## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ಭಾಗೋಜಿಕೊಪ್ಪ ಗ್ರಾಮದ ಹದ್ದಿನಲ್ಲಿ ಬಸಿ ನೀರಿನ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ಪತ್ರ ಸಂಖ್ಯೆ : ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011–12/4402, ದಿನಾಂಕ : 20–08–2011.

**ಪ್ರಸ್ತಾವನೆ :**

ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ಭಾಗೋಜಿಕೊಪ್ಪ ಗ್ರಾಮದ ಹದ್ದಿನಲ್ಲಿ ಬಸಿ ನೀರಿನ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಭಾಗೋಜಿಕೊಪ್ಪ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ದಿನಾಂಕ : 20–08–2011ರ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ.

ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರ ಅಧಿಸೂಚನೆಯನ್ನು ದಿನಾಂಕ : 27–12–07ರಂದು ಹೊರಡಿಸಿದೆ. ಭೂಸ್ವಾಧೀನಾಧಿಕಾರಿಗಳು ದಿನಾಂಕ : 15–06–09ರಂದು ರಚಿಸಿದ ಐತೀರ್ಪಿನಲ್ಲಿ ಪ್ರತಿ ಎಕರೆಗೆ ರೂ. 24,000/–ಗಳ ಮಾರುಕಟ್ಟೆ ಬೆಲೆ ನಿಗದಿಪಡಿಸಿರುತ್ತಾರೆ. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ರಾಮದುರ್ಗ ಸಿವಿಲ್ (ಹಿರಿಯ ವಿಭಾಗ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣಗಳನ್ನು ದಾಖಲಿಸಿದ್ದು, ನ್ಯಾಯಾಲಯವು ಪ್ರತಿ ಎಕರೆಗೆ ರೂ. 2,60,000/–ಗಳನ್ನು ನಿಗದಿಪಡಿಸಿದೆ. ಸಿವಿಲ್ ನ್ಯಾಯಾಲಯದ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯು ಪತ್ರ ಸಂಖ್ಯೆ : ಆರ್‌ಡಿ 1446 ಎಲ್‌ಸಿಬಿ 2011, 02–01–12ರಲ್ಲಿ ಅಭಿಪ್ರಾಯ ನೀಡಿದೆ. ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ :

| ಕ್ರ. ಸಂ. | ಎಲ್‌ಎಸಿ | ಭಾಗೋಜಿಕೊಪ್ಪ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 10/10 | 65/3, 66/3 | 2–36 | 1085837 |
| 2 | 11/10 | 66/1ಪಿ2 | 0–33 | 309260 |
| 3 | 12/10 | 66/2 | 1–01 | 384110 |
| 4 | 13/10 | 66/4 | 1–14 | 505743 |
| 5 | 14/10 | 66/5 | 0–30 | 281190 |
| 6 | 15/10 | 67/2 | 0–09 | 84707 |
| 7 | 16/10 | 67/3ಎ+3ಬಿ | 0–10 | 94063 |
| 8 | 17/10 | 67/5 | 0–29 | 271834 |
| | **ಒಟ್ಟು** | | | **3016744** |

ಪ್ರಸ್ತಾವನೆಯಲ್ಲಿನ ಅಂಶಗಳನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ : ಸನೀಇ 118 ಭೂಸ್ವಾಪ್ರ 2011, ಬೆಂಗಳೂರು, ದಿನಾಂಕ : 30–03–2012**

ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ಭಾಗೋಜಿಕೊಪ್ಪ ಗ್ರಾಮದ ಹದ್ದಿನಲ್ಲಿ ಬಸಿ ನೀರಿನ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಭಾಗೋಜಿಕೊಪ್ಪ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ರೂ. 30,16,744–00 ಗಳನ್ನು (ಮೂವತ್ತು ಲಕ್ಷದ ಹದಿನಾರು ಸಾವಿರದ ಏಳುನೂರ ನಲವತ್ತ ನಾಲ್ಕು ರೂ.ಗಳು ಮಾತ್ರ) ಪಾವತಿಸಲು ಸರ್ಕಾರ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 30,16,744/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕ ಪ್ರತ್ಯಾಯೋಜನೆಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಪಿ.ಆರ್. 1101 ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೆಳಗಾಂ ಜಿಲ್ಲೆ, ಹುಕ್ಕೇರಿ ತಾಲ್ಲೂಕು ಬೆಳವಿ ಗ್ರಾಮದ ಕೆರೆ ನಿರ್ಮಾಣಕ್ಕಾಗಿ (ಹೆಚ್ಚುವರಿ ಕ್ಷೇತ್ರ) ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ಪತ್ರ ಸಂಖ್ಯೆ : ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011–12/6662, ದಿನಾಂಕ : 30–12–2011.

**ಪ್ರಸ್ತಾವನೆ :**

ಬೆಳಗಾಂ ಜಿಲ್ಲೆ, ಹುಕ್ಕೇರಿ ತಾಲ್ಲೂಕು ಬೆಳವಿ ಗ್ರಾಮದ ಕೆರೆ ನಿರ್ಮಾಣಕ್ಕಾಗಿ (ಹೆಚ್ಚುವರಿ ಕ್ಷೇತ್ರ) ಸ್ವಾಧೀನಪಡಿಸಿಕೊಳ್ಳಲಾದ ಬೆಳವಿ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ದಿನಾಂಕ : 30–12–2011ರ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ.

ಪ್ರಸ್ತಾಪಿಸಿರುವ ಬೆಳವಿ ಗ್ರಾಮದ ಹದ್ದಿಯಲ್ಲಿ ಬರುವ ಹುಕ್ಕೇರಿ ತಾಲ್ಲೂಕಿನ ಬೆಳವಿ ಗ್ರಾಮಕ್ಕೆ ಸೇರಿದ ಒಟ್ಟು 3–09 ಎಕರೆ ಜಮೀನನ್ನು ಹೆಚ್ಚುವರಿಯಾಗಿ ಭೂಸ್ವಾಧೀನಪಡಿಸಿಕೊಳ್ಳಲಾಗಿದ್ದು, 4(1)ರ ಅಧಿಸೂಚನೆಯನ್ನು ದಿನಾಂಕ 22–03–1990, 6(1)ರ ಅಧಿಸೂಚನೆಯನ್ನು ದಿನಾಂಕ 14–02–1991 ರಂದು ಹೊರಡಿಸಲಾಗಿದೆ. ಭೂಸ್ವಾಧೀನಾಧಿಕಾರಿಗಳು ಐತೀರ್ಪನ್ನು ದಿನಾಂಕ 11–02–1993ರಂದು ಹೊರಡಿಸಿರುತ್ತಾರೆ. ಸದರಿ ಗ್ರಾಮದ ಜಮೀನನ್ನು ದಿನಾಂಕ : 03–02–1991ರಲ್ಲಿ ಕಬ್ಜೆ ಪಡೆಯಲಾಗಿದೆ.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಪಡೆದ ಭೂಮಾಲೀಕರು ಹೆಚ್ಚುವರಿ ಪರಿಹಾರ ಧನಕ್ಕಾಗಿ ಹುಕ್ಕೇರಿ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ದಾಖಲಿಸಿದ್ದ ಎಲ್.ಎ.ಸಿ. ಪ್ರಕರಣ ಸಂಖ್ಯೆ : 45/04ನ್ನು ದಾಖಲಿಸಿದ್ದು, ಮಾನ್ಯ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನ ಪಾವತಿಸಲು ದಿನಾಂಕ 15–04–2004ರ ಆದೇಶದಲ್ಲಿ ಪ್ರತಿ ಎಕರೆ ಜಮೀನಿಗೆ ರೂ. 1,30,000/–ಗಳನ್ನು ನಿಗದಿಪಡಿಸಿ ತೀರ್ಪು ನೀಡಿದೆ. ಸಿವಿಲ್ ನ್ಯಾಯಾಲಯದ ತೀರ್ಪಿಗೆ ತೃಪ್ತರಾಗದ ಭೂಮಾಲೀಕರು ಮಾನ್ಯ ಉಚ್ಚ ನ್ಯಾಯಾಲಯದಲ್ಲಿ ಮೇಲ್ಮನವಿ ಎಂಎಫ್‌ಎ 7577/04ನ್ನು ದಾಖಲಿಸಿದ್ದು, ಮಾನ್ಯ ನ್ಯಾಯಾಲಯವು ದಿನಾಂಕ : 23–02–07ರಂದು ನೀಡಿದ ತೀರ್ಪಿನಲ್ಲಿ ಸಿವಿಲ್ ನ್ಯಾಯಾಲಯದ ಆದೇಶವನ್ನು ಎತ್ತಿ ಹಿಡಿದು, ಸದರಿ ಮೇಲ್ಮನವಿಯನ್ನು ವಜಾಗೊಳಿಸಿದೆ.

ಉಚ್ಚ ನ್ಯಾಯಾಲಯದ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯ ಮುಖ್ಯಸ್ಥರು ಹಾಗೂ ಪದನಿಮಿತ್ತದ ಸರ್ಕಾರದ ಉಪ ಕಾರ್ಯದರ್ಶಿಯವರು (ವ್ಯಾಜ್ಯ–VI) ಇವರ ಪತ್ರ ಸಂಖ್ಯೆ : ಲಾ 1478 ಎಲ್‌ಬಿಎಸ್ 2007, ದಿನಾಂಕ : 17–10–07ರಂದು ಅಭಿಪ್ರಾಯ ನೀಡಿದೆ.

ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ ;

| ಕ್ರ. ಸಂ. | ಎಲ್ಎಸಿ | ಎಂಎಫ್‌ಎ ಸಂಖ್ಯೆ | ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 45/04 | 7577/04 | 428 | 3–09 | 13,40,692–00 |
| **ಒಟ್ಟು** | | | | | **13,40,692–00** |

ಪ್ರಸ್ತಾವನೆಯಲ್ಲಿನ ಅಂಶಗಳನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ : ಸನೀಇ 13 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ : 30–03–2012**

ಬೆಳಗಾಂ ಜಿಲ್ಲೆ, ಹುಕ್ಕೇರಿ ತಾಲ್ಲೂಕು ಬೆಳವಿ ಗ್ರಾಮದ ಹದ್ದಿನಲ್ಲಿ ಬಸಿ ನೀರಿನ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಬೆಳವಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್ 428ರ ಜಮೀನಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ರೂ. 13,40,692–00 ಗಳನ್ನು (ಹದಿಮೂರು ಲಕ್ಷದ ನಲವತ್ತು ಸಾವಿರದ ಆರುನೂರ ತೊಂಭತ್ತೆರಡು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 13,40,692/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕ ಪ್ರತ್ಯಾಯೋಜನೆಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

ಪಿ.ಆರ್. 1102

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೀದರ್ ಜಿಲ್ಲೆ, ಔರಾದ್ ತಾಲ್ಲೂಕು ಆಲೂರು-ಬೇಲೂರು ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ : 02-11-2011ರ ಪತ್ರದ ಸಂಖ್ಯೆ : ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011-12/5586.

**ಪ್ರಸ್ತಾವನೆ :**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಬೀದರ್ ಜಿಲ್ಲೆ, ಔರಾದ್ ತಾಲ್ಲೂಕು ಆಲೂರು-ಬೇಲೂರು ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಶೇಂಬಳ್ಳಿ ಗ್ರಾಮದ ಸರ್ವೆ ನಂಬರ್‌ಗಳಿಗೆ ಸೇರಿದ ಜಮೀನುಗಳಿಗೆ ಬೀದರ್ ಸಿವಿಲ್ ನ್ಯಾಯಾಲಯವು (ಹಿರಿಯ ಶ್ರೇಣಿ) ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ :

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ : 25-05-2000.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ : 30-04-2002.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಲ್ಲಿ ಸೇರಿದ್ದ ಕೆಲವೊಂದು ಸ.ನಂ.ಗಳ ಭೂಮಾಲೀಕರು ಹೆಚ್ಚಿನ ಪರಿಹಾರ ಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಬೀದರ್‌ನ ಹಿರಿಯ ಶ್ರೇಣಿ ಸಿವಿಲ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಎಲ್.ಎ.ಸಿ ಪ್ರಕರಣ ಸಂಖ್ಯೆ : 22/06ನ್ನು ದಾಖಲಿಸಿದ್ದು, ನ್ಯಾಯಾಲಯವು ದಿನಾಂಕ : 18-04-2009ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ಜಮೀನಿಗೆ ರೂ. 1,01,700/-ಗಳ ಭೂಮೌಲ್ಯ ನಿಗದಿಪಡಿಸಿದೆ. ಈ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸುವ ಅಗತ್ಯವಿಲ್ಲವೆಂದು ಕಂದಾಯ ಇಲಾಖೆ (ಎಲ್‌ಎಸಿ)ಯ ಪತ್ರ ಸಂಖ್ಯೆ : ಆರ್‌ಡಿ 214 ಎಲ್‌ಸಿಜಿ 2011, ದಿನಾಂಕ : 18-06-2011ರಲ್ಲಿ ಅಭಿಪ್ರಾಯ ನೀಡಲಾಗಿದೆ. ಪಾವತಿಸಬೇಕಾದ ಹೆಚ್ಚಿನ ಪರಿಹಾರ ಧನದ ವಿವರ ಕೆಳಕಂಡಂತಿದೆ :

| ಕ್ರ. ಸಂ. | ಎಲ್‌ಎಸಿ | ಸ.ನಂ. | ವಿಸ್ತೀರ್ಣ ಎ-ಗುಂ | ಗ್ರಾಮ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 22/05 | 12/6-12 | 5-34 | ಶೇಂಬಳ್ಳಿ | 17,63,460-00 |
| ಒಟ್ಟು | | | | | **17,63,460-00** |

- **ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.**

ಪ್ರಸ್ತಾವನೆಯನ್ನು ಪರಿಶೀಲಿಸಿ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ : ಸನೀಇ 174 ಭೂಸ್ವಾಪ್ರ 2011, ಬೆಂಗಳೂರು, ದಿನಾಂಕ : 30-03-2012**

ಬೀದರ್ ಜಿಲ್ಲೆ, ಔರಾದ್ ತಾಲ್ಲೂಕು ಆಲೂರು-ಬೇಲೂರು ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಶೇಂಬಳ್ಳಿ ಗ್ರಾಮಕ್ಕೆ ಸೇರಿದ 12/6-12ರ ಸರ್ವೆ ನಂಬರ್‌ಗೆ ಸೇರಿದ ಜಮೀನುಗಳಿಗೆ ಬೀದರ್‌ನ ಹಿರಿಯ ಶ್ರೇಣಿ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿರುವ ತೀರ್ಪಿನಂತೆ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕ ಹಾಕಿದ ಪರಿಹಾರ ಧನ ಮೊತ್ತ ರೂ. 17,63,460-00 ಗಳನ್ನು (ಹದಿನೇಳು ಲಕ್ಷದ ಅರವತ್ತಮೂರು ಸಾವಿರದ ನಾನೂರ ಅರವತ್ತು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011-12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702-00-800-1-00-ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು-ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 17,63,460/-ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20-10-2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಪಿ.ಆರ್. 1103 ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಕೊಪ್ಪಳ ಜಿಲೆ ಮತ್ತು ತಾಲ್ಲೂಕಿನ ಚಳ್ಳಾರಿ ಜಿನುಗು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ : 28–09–2011ರ ಪತ್ರ ಸಂಖ್ಯೆ : ಮುಇಂ/ಸನೀ(ಉ)/ಭೂಸ್ವಾಪ್ರ/2011–12/5029.

**ಪ್ರಸ್ತಾವನೆ :**

ಕೊಪ್ಪಳ ಜಿಲೆ ಮತ್ತು ತಾಲ್ಲೂಕಿನ ಚಳ್ಳಾರಿ ಜಿನುಗು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಚಳ್ಳಾರಿ ಗ್ರಾಮದ ಜಮೀನುಗಳಿಗೆ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ಕೊಪ್ಪಳ ಇವರು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ ಓದಲಾದ ದಿನಾಂಕ : 28–09–2011ರ ಪತ್ರದಲ್ಲಿ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ :

– ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ : 04–08–2005.
– ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ : 22–05–2008. ಜಿಲ್ಲಾಧಿಕಾರಿಗಳು, ಕೊಪ್ಪಳ ಆದೇಶ ದಿನಾಂಕ : 18–06–2008.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳದ ಸಿವಿಲ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಭೂಸ್ವಾಧೀನ ಪ್ರಕರಣಗಳನ್ನು ದಾಖಲಿಸಿದ್ದು, ಈ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ಪ್ರತಿ ಎಕರೆಗೆ ರೂ. 1,53,000/–ಗಳಿಗೆ ಹೆಚ್ಚಿಸಿ ಪರಿಹಾರಕ್ಕೆ ತೀರ್ಪು ನೀಡಿದೆ. ಈ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯು ಪತ್ರ ಸಂಖ್ಯೆ : ಆರ್‌ಡಿ 210 ಎಲ್‌ಸಿಜಿ 2011, ದಿನಾಂಕ : 18–06–2011ರಲ್ಲಿ ಅಭಿಪ್ರಾಯ ನೀಡಿದೆ.

ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ :

| ಕ್ರ. ಸಂ. | ಎಲ್‌ಎಸಿ ಸಂಖ್ಯೆ | ಸ.ನಂ. | ಗ್ರಾಮ | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 4/10 | 56 | ಚಳ್ಳಾರಿ | 1–00 | 3,82,440–00 |
| **ಒಟ್ಟು** | | | | | **3,82,440–00** |

**ಸರ್ಕಾರಿ ಆದೇಶ ಸಂಖ್ಯೆ : ಸನೀಇ 151 ಭೂಸ್ವಾಪ್ರ 2011, ಬೆಂಗಳೂರು, ದಿನಾಂಕ : 31–03–2012**

ಕೊಪ್ಪಳ ಜಿಲ್ಲೆ ಮತ್ತು ತಾಲ್ಲೂಕಿನ ಚಳ್ಳಾರಿ ಜಿನುಗು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಚಳ್ಳಾರಿ ಗ್ರಾಮದ ಮೇಲ್ಕಂಡ ಸರ್ವೆ ನಂಬರ್ ಜಮೀನುಗಳಿಗೆ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ಕೊಪ್ಪಳ ಇವರು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರ ಮೊತ್ತ ರೂ. 3,82,440–00ಗಳನ್ನು (ಮೂರು ಲಕ್ಷದ ಎಂಭತ್ತೆರಡು ಸಾವಿರದ ನಾನೂರ ನಲವತ್ತು ರೂ.ಗಳು ಮಾತ್ರ) ಪಾವತಿಸಲು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 3,82,440/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ
**ಕೆ.ಸಿ. ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

ಪಿ.ಆರ್. 1104

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕಿನ ರಾಯನಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ : 18-11-2011ರ ಪತ್ರ ಸಂಖ್ಯೆ : ಮುಇಂ/ಸನೀ(ಉ)ವ/ಭೂಸ್ವಾಪ್ರ/2011-12/5813.

**ಪ್ರಸ್ತಾವನೆ :**

ಕೊಪ್ಪಳ ಜಿಲ್ಲೆ ಕುಷ್ಟಗಿ ತಾಲ್ಲೂಕಿನ ರಾಯನಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ತಾವರಗೇರಾ ಗ್ರಾಮದ ಜಮೀನುಗಳಿಗೆ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ಕೊಪ್ಪಳ ಇವರು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ ಓದಲಾದ ದಿನಾಂಕ : 18-11-2011ರ ಪತ್ರದಲ್ಲಿ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ :

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ : 01-02-1996.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ : 20-02-2001.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳದ ಸಿವಿಲ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಎಲ್.ಎ.ಸಿ ಪ್ರಕರಣ ಸಂಖ್ಯೆ : 50/02ನ್ನು ದಾಖಲಿಸಿದ್ದು, ಮಾನ್ಯ ನ್ಯಾಯಾಲಯವು ದಿನಾಂಕ : 26-09-2006ರಂದು ನೀಡಿದ ಆದೇಶದಲ್ಲಿ ಸ್ವಾಧೀನಪಡಿಸಿಕೊಂಡ ಜಮೀನುಗಳ ಮಾರುಕಟ್ಟೆ ಬೆಲೆಯನ್ನು ಪ್ರತಿ ಎಕರೆಗೆ ರೂ. 95,000/-ಗಳನ್ನು ನಿಗದಿಪಡಿಸಿ ಈ ಮೊತ್ತದ ಮೇಲೆ ಇತರೆ ಸವಲತ್ತುಗಳನ್ನು ನೀಡುವಂತೆ ಆದೇಶಿಸಿದೆ. ಸಿವಿಲ್ ನ್ಯಾಯಾಲಯದ ತೀರ್ಪಿಗೂ ಸಹ ತೃಪ್ತರಾಗದ ಭೂಮಾಲೀಕರು ಉಚ್ಛ ನ್ಯಾಯಾಲಯದಲ್ಲಿ ಎಂ.ಎಫ್.ಎ. ಸಂಖ್ಯೆ : 520/07ನ್ನು ದಾಖಲಿಸಿರುತ್ತಾರೆ. ಮಾನ್ಯ ಉಚ್ಛ ನ್ಯಾಯಾಲಯವು ದಿನಾಂಕ : 20-07-2007ರಂದು ನೀಡಿದ ತೀರ್ಪಿನಲ್ಲಿ ವಜಾಗೊಳಿಸಿದೆ. ಈ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯು ಪತ್ರ ಸಂಖ್ಯೆ ಲಾ : 2558 ಎಲ್‌ಎಸ್‌ಪಿ 07 ದಿನಾಂಕ : 04-01-2008ರಲ್ಲಿ ಅಭಿಪ್ರಾಯ ನೀಡಿದೆ.

ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ :

| ಕ್ರ. ಸಂ. | ಎಲ್‌ಎಸಿ ಸಂಖ್ಯೆ | ಎಂಎಫ್‌ಎ ಸಂಖ್ಯೆ | ತಾವರಗೇರಾ ಗ್ರಾಮದ ಸ.ನಂ. | ವಿಸ್ತೀರ್ಣ ಎ-ಗುಂ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 50/02 | 520/07 | 265,265/2 | 1-24 | 10,01,528-00 |
| **ಒಟ್ಟು** | | | | | **10,01,528-00** |

**ಸರ್ಕಾರಿ ಆದೇಶ ಸಂಖ್ಯೆ : ಸನೀಇ 177 ಭೂಸ್ವಾಪ್ರ 2011, ಬೆಂಗಳೂರು, ದಿನಾಂಕ : 31-03-2012**

ಕೊಪ್ಪಳ ಜಿಲ್ಲೆ ಕುಷ್ಟಗಿ ತಾಲ್ಲೂಕಿನ ರಾಯನಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ತಾವರಗೇರಾ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ಕೊಪ್ಪಳ ಇವರು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರ ಮೊತ್ತ ರೂ. 10,01,528-00ಗಳನ್ನು (ಹತ್ತು ಲಕ್ಷದ ಒಂದು ಸಾವಿರದ ಐನೂರ ಇಪ್ಪತ್ತೆಂಟು ರೂ.ಗಳು ಮಾತ್ರ) ಪಾವತಿಸಲು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011-12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702-00-800-1-00-ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು-ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 10,01,528/-ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20-10-2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಅಧಿಕಾರ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

ಪಿ.ಆರ್. 1105

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಗುಲ್ಬರ್ಗಾ ಜಿಲ್ಲೆ, ಚಿಂಚೋಳಿ ತಾಲ್ಲೂಕು ಹಸರಗುಂಡಗಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ: ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011-12/5583, ದಿನಾಂಕ: 02-11-2011.

**ಪ್ರಸ್ತಾವನೆ:-**

ಗುಲ್ಬರ್ಗಾ ಜಿಲ್ಲೆ, ಚಿಂಚೋಳಿ ತಾಲ್ಲೂಕು ಹೆಸರಗುಂಡಗಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಗುರಂಪಳ್ಳಿ ಮತ್ತು ಹಸರಗುಂಡಗಿ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣದಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 04-12-2003.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 12-09-2006.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಚಿಂಚೋಳಿ ಸಿವಿಲ್ (ಹಿರಿಯ ವಿಭಾಗ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣಗಳನ್ನು ದಾಖಲಿಸಿದ್ದು, ನ್ಯಾಯಾಲಯವು ಎಲ್.ಎ.ಸಿ. ಸಂಖ್ಯೆ: 53/08 ಮತ್ತು 22/08ರಲ್ಲಿ ನೀಡಿದ ಆದೇಶದಲ್ಲಿ ಪ್ರತಿ ಎಕರೆಗೆ ರೂ. 1,44,000/-ಗಳು ಹಾಗೂ ಎಲ್.ಎ.ಸಿ. ಸಂಖ್ಯೆ: 59/08 ಮತ್ತು 60/08 ರಲ್ಲಿ ಪ್ರತಿ ಎಕರೆಗೆ ರೂ. 96,000/- ಗಳನ್ನು ಮತ್ತು ಎಲ್.ಎ.ಸಿ. ಸಂಖ್ಯೆ: 56/08, ದಿನಾಂಕ 24-10-2008 ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ರೂ. 1,21, 500/- ಗಳನ್ನು ನಿಗದಿಪಡಿಸಿ ಇತರೆ ಸವಲತ್ತುಗಳೊಂದಿಗೆ ಪಾವತಿಸಲು ಆದೇಶಿಸಿದೆ. ಈ ಆದೇಶಗಳ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶವು ಪತ್ರ ಸಂಖ್ಯೆ: ಆರ್‌ಡಿ 1142 ಎಲ್‌ಸಿಜಿ 10, ಆರ್‌ಡಿ 1143 ಎಲ್‌ಸಿಜಿ 10 ಮತ್ತು ಆರ್‌ಡಿ 1126 ಎಲ್‌ಸಿಜಿ 10, ದಿನಾಂಕ 31-12-2010ರ ಪತ್ರಗಳಲ್ಲಿ ಅಭಿಪ್ರಾಯ ನೀಡಿದೆ.

ಪಾವತಿಸಬೇಕಾದ ಪರಿಹಾರದ ವಿವರ ಕೆಳಕಂಡಂತಿದೆ:

| ಕ್ರ. ಸಂ. | ಎಲ್‌ಎಸಿ ಸಂಖ್ಯೆ | ಸ.ನಂ. | ಗ್ರಾಮ | ವಿಸ್ತೀರ್ಣ ಎ-ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ |
|---|---|---|---|---|---|
| 1 | 53/08 | 52/2 | ಗುರಂಪಳ್ಳಿ | 0-16 | 115560 |
| 2 | 59/08 | 44 | ಗುರಂಪಳ್ಳಿ | 2-05 | 408507 |
| 3 | 60/08 | 45/3 | ಗುರಂಪಳ್ಳಿ | 0-01 | 5103 |
| 4 | 22/08 | 23/1-3 | ಹಸರಗುಂಡಗಿ | 1-33 | 482400 |
| 5 | 56/08 | 47/2ಸಿ | ಗುರಂಪಳ್ಳಿ | 1-08 | 273024 |
| | | | | **ಒಟ್ಟು** | **1284594** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 156 ಭೂಸ್ವಾಪ್ರ 2011**

**ಬೆಂಗಳೂರು, ದಿನಾಂಕ : 30ನೇ ಮಾರ್ಚ್ 2012.**

ಗುಲ್ಬರ್ಗಾ ಜಿಲ್ಲೆ, ಚಿಂಚೋಳಿ ತಾಲ್ಲೂಕು ಹಸರಗುಂಡಗಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಗುರಂಪಳ್ಳಿ ಮತ್ತು ಹಸರಗುಂಡಗಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸ.ನಂ. ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ. 12,84,594/- ಗಳನ್ನು (ಹನ್ನೆರಡು ಲಕ್ಷದ ಎಂಭತ್ತ್ನಾಲ್ಕು ಸಾವಿರದ ಐನೂರ ತೊಂಭತ್ತ್ನಾಲ್ಕು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011-12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702-00-800-1-00- ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು- ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 12,84,594/- ಗಳನ್ನು ಹಂಚಿಕೆ ಮಾಡಿ, ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

ಪಿ.ಆರ್. 1106

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ :** ಉತ್ತರ ಕನ್ನಡ ಜಿಲ್ಲೆ ಜೋಯಿಡಾ ತಾಲ್ಲೂಕಿನ ರಾಮನಗರ ಹತ್ತಿರ ಪಂಡರಿ ನದಿಗೆ ಅಡ್ಡಲಾಗಿ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣ ಕಾಮಗಾರಿಯ ಅಂದಾಜು ಪಟ್ಟಿಗೆ ಆಡಳಿತಾತ್ಮಕ ಅನುಮೋದನೆ ನೀಡುವ ಬಗ್ಗೆ.

**ಓದಲಾಗಿದೆ :** ದಿನಾಂಕ 20–03–2012ರ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ಪತ್ರ ಸಂಖ್ಯೆ: ಮುಇಂ/ಸನೀ(ಉ)ವ/ಬಿಜೆಪಿ/ ಎಇ/2/2011–12/1597 ದಿನಾಂಕ: 20–03–2012.

**ಪ್ರಸ್ತಾವನೆ:–**

ಉತ್ತರ ಕನ್ನಡ ಜಿಲ್ಲೆ ಜೋಯಿಡಾ ತಾಲ್ಲೂಕಿನ ರಾಮನಗರ ಹತ್ತಿರ ಪಂಡರಿ ನದಿಗೆ ಅಡ್ಡಲಾಗಿ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣ ಕಾಮಗಾರಿಯ 2011–12ನೇ ಸಾಲಿಗೆ ಮುಂದುವರೆಸಲಾದ 2010–11ನೇ ಸಾಲಿನ ದರಪಟ್ಟಿಯಂತೆ ತಯಾರಿಸಲಾದ ರೂ. 268.00 ಲಕ್ಷಗಳ ಅಂದಾಜು ಪಟ್ಟಿಗೆ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರರವರು ಮೇಲೆ ಓದಲಾದ ಪತ್ರದಲ್ಲಿ ಆಡಳಿತಾತ್ಮಕ ಅನುಮೋದನೆ ಕೋರಿ ಪ್ರಸ್ತಾವನೆ ಸಲ್ಲಿಸಿದ್ದಾರೆ.

ಪ್ರಸ್ತಾಪಿತ ಬ್ಯಾರೇಜಿನ ಉದ್ದ 64.00ಮಿ., ಎತ್ತರ 3.50ಮೀ. ಆಗಿದ್ದು 12 ಮುಖ್ಯ ನಡುಗಂಬಗಳು ಹಾಗೂ 13 ನೆಪಮಾತ್ರ ನಡುಗಂಬ ಗಳೊಂದಿಗೆ ನಿರ್ಮಿಸಲು ಅಂದಾಜಿನಲ್ಲಿ ವಿನ್ಯಾಸಿಸಿದೆ. ಈ ಬ್ಯಾರೇಜ್‌ನ ಶೇಖರಣಾ ಸಾಮರ್ಥ್ಯ 10.84 ದಶಲಕ್ಷ ಘನ ಅಡಿಗಳಾಗಿದ್ದು 124ಹೆ. ಪ್ರದೇಶಕ್ಕೆ ನೀರಾವರಿ ಸೌಲಭ್ಯ ಕಲ್ಪಿಸಲು ಉದ್ದೇಶಿಸಿದೆ. ಈ ಯೋಜನೆಯ ಲಾಭ ವೆಚ್ಚದ ಅನುಪಾತವು ಶೇ. 10ರ ದರದಲ್ಲಿ 2.61 ಆಗಿದ್ದು ಆರ್ಥಿಕವಾಗಿ ಶಕ್ಯವಾಗಿರುತ್ತದೆ.

ಈ ಕಾಮಗಾರಿಯ ಅಂದಾಜಿಗೆ 2011–12ನೇ ಸಾಲಿನ ಲೆಕ್ಕಶೀರ್ಷಿಕೆ "4702–00–10–5–01–139 ಆಣೆಕಟ್ಟು ಮತ್ತು ಪಿಕಪ್‌ಗಳ ನಿರ್ಮಾಣ–ಪ್ರಧಾನ ಕಾಮಗಾರಿಗಳು ರಡಿ ಆಡಳಿತಾತ್ಮಕ ಅನುಮೋದನೆ ನೀಡಲು ಪರಿಗಣಿಸಿದೆ.

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 50 ಅಪಿಬಿಂ (ತಾಂತ್ರಿಕ) 2012**

**ಬೆಂಗಳೂರು, ದಿನಾಂಕ : 29ನೇ ಮಾರ್ಚ್ 2012.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಉತ್ತರ ಕನ್ನಡ ಜಿಲ್ಲೆ ಜೋಯಿಡಾ ತಾಲ್ಲೂಕಿನ ರಾಮನಗರ ಹತ್ತಿರ ಪಂಡರಿ ನದಿಗೆ ಅಡ್ಡಲಾಗಿ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣ ಕಾಮಗಾರಿಯ 2011–12ನೇ ಸಾಲಿಗೆ ಮುಂದುವರೆಸಲಾದ 2010–11ನೇ ಸಾಲಿನ ದರಪಟ್ಟಿಯಂತೆ ತಯಾರಿಸಲಾದ ರೂ.268.00 ಲಕ್ಷಗಳ (ಎರಡು ಕೋಟಿ ಅರವತ್ತೆಂಟು ಲಕ್ಷ ಮಾತ್ರ) ಅಂದಾಜು ಪಟ್ಟಿಗೆ ಕೆಳಕಂಡ ಷರತ್ತಿಗೊಳಪಟ್ಟು ಸರ್ಕಾರವು ಆಡಳಿತಾತ್ಮಕ ಅನುಮೋದನೆ ನೀಡಿದೆ.

1) ಕಾಮಗಾರಿಯ ವೆಚ್ಚವು ಯಾವುದೇ ಕಾರಣಕ್ಕೂ ಅನುಮೋದಿಸಿದ ಟೆಂಡರ್ ಮೊತ್ತಕ್ಕಿಂತ ಹೆಚ್ಚಾಗಬಾರದು ಹಾಗೂ ಕಾಮಗಾರಿಯನ್ನು ಕಾಲಮಿತಿಯೊಳಗೆ ಪೂರ್ಣಗೊಳಿಸತಕ್ಕದ್ದು.
2) ಒಂದುವೇಳೆ ಸ್ಥಳ ಪರಿಸ್ಥಿತಿಗೆ ಅನುಗುಣವಾಗಿ ಹೆಚ್ಚಳ ನಿರೀಕ್ಷಿಸಿದಲ್ಲಿ ತಕ್ಷಣವೇ ಸಕ್ಷಮ ಪ್ರಾಧಿಕಾರದಿಂದ ಅನುಮೋದನೆ ಪಡೆದು ಕಾಮಗಾರಿಯನ್ನು ಪೂರ್ಣಗೊಳಿಸತಕ್ಕದ್ದು.
3) ಕಾಮಗಾರಿ ಪ್ರಾರಂಭಿಸುವ ಮುನ್ನ ವಿನ್ಯಾಸ ಬದಲಾವಣೆಯಿಂದಾಗಿ ಅಥವಾ ಬೇರೆ ಕಾರಣದಿಂದ ಅನುಮೋದಿಸಿದ ಅಂದಾಜು ಮೊತ್ತ ಹೆಚ್ಚಾಗುವ ಸಂಭವ ಇದ್ದಲ್ಲಿ, ತಕ್ಷಣ ಪರಿಷ್ಕೃತ ಅಂದಾಜಿಗೆ ಸಕ್ಷಮ ಪ್ರಾಧಿಕಾರದಿಂದ ಅನುಮೋದನೆ ಪಡೆದು ನಂತರ ಕಾಮಗಾರಿಯನ್ನು ಪ್ರಾರಂಭಿಸುವುದು.
4) ಕಾಮಗಾರಿಯ ಅಂದಾಜು ಪಟ್ಟಿಗೆ ತಾಂತ್ರಿಕ ಮೌಲ್ಯ ನಿರ್ಣಯ ಸಮಿತಿ/ತಾಂತ್ರಿಕ ಸಮಿತಿಯ ತೀರುವಳಿ ಪಡೆಯುವುದು.
5) ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮ 1999ರ ಅನುಸಾರ ಟೆಂಡರ್ ಕರೆದು ತೆಗೆದುಕೊಳ್ಳತಕ್ಕದ್ದು.
6) ಇ.ಐ.ಆರ್.ಎಲ್/ವರ್ಕ್‌ಸ್ಲಿಪ್‌ಗಳನ್ನು ಸಲ್ಲಿಸಬೇಕಾದಲ್ಲಿ ತಕ್ಷಣವೇ ಸಲ್ಲಿಸತಕ್ಕದ್ದು.
7) ತಾಂತ್ರಿಕ ಮಂಜೂರಾತಿಯನ್ನು ನೀಡುವ ಮೊದಲು ಅಂದಾಜನ್ನು ಮತ್ತೊಮ್ಮೆ ವಿವರವಾಗಿ ಪರಿಶೀಲಿಸುವುದು.
8) ಈ ಯೋಜನೆಗೆ ನೀರು ಬಳಕೆದಾರರ ಸಂಘನ್ನು ಸೃಜಿಸುವುದು.

ಈ ಆದೇಶವನ್ನು ಸರ್ಕಾರದ ಆದೇಶ ಸಂಖ್ಯೆ: ಎಫ್‌ಡಿ. 1 ಟಿ.ಎಫ್.ಪಿ 2008 ದಿನಾಂಕ: 16–05–2008ರಲ್ಲಿ ಇಲಾಖಾ ಕಾರ್ಯದರ್ಶಿಗಳಿಗೆ ಪ್ರತ್ಯಾಯೋಜಿಸಿರುವ ಅಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲ ಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

ಪಿ.ಆರ್. 1107

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ :** ಹಾವೇರಿ ಜಿಲ್ಲೆ ಹಾನಗಲ್ ತಾಲ್ಲೂಕಿನ ಮಕರವಳ್ಳಿ ಗ್ರಾಮದ ಹತ್ತಿರ ವರದಾ ನದಿಗೆ ಅಡ್ಡಲಾಗಿ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣ ಕಾಮಗಾರಿಯ ಅಂದಾಜು ಪಟ್ಟಿಗೆ ಆಡಳಿತಾತ್ಮಕ ಅನುಮೋದನೆ ನೀಡುವ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ಪತ್ರ ಸಂಖ್ಯೆ: ಮುಇಂ/ಸನೀ(ಉ)ವಲಯ/ಬಿಜೆಪಿ/ ಎಇ–3/2011–12.

**ಪ್ರಸ್ತಾವನೆ:–**

ಹಾವೇರಿ ಜಿಲ್ಲೆ ಹಾನಗಲ್ ತಾಲ್ಲೂಕಿನ ಮಕರವಳ್ಳಿ ಗ್ರಾಮದ ಹತ್ತಿರ ವರದಾ ನದಿಗೆ ಅಡ್ಡಲಾಗಿ ಬ್ಯಾರೇಜ್ ನಿರ್ಮಾಣ ಕಾಮಗಾರಿಯ 2011–12ನೇ ಸಾಲಿಗೆ ಮುಂದುವರೆಸಿರುವ 2010–11ನೇ ಸಾಲಿನ ದರಪಟ್ಟಿಯಂತೆ ತಯಾರಿಸಲಾದ ರೂ. 4,99,98,832.00 ಗಳ ಅಂದಾಜು ಪಟ್ಟಿಗೆ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರರವರು ಮೇಲೆ ಓದಲಾದ ಪತ್ರದಲ್ಲಿ ಆಡಳಿತಾತ್ಮಕ ಅನುಮೋದನೆ ಕೋರಿ ಪ್ರಸ್ತಾವನೆ ಸಲ್ಲಿಸಿದ್ದಾರೆ.

ಪ್ರಸ್ತಾಪಿತ ಬ್ಯಾರೇಜಿನ ಉದ್ದ 128.80ಮೀ., ಎತ್ತರ 4.00ಮೀ. ಮತ್ತು ಮೇಲ್ಭಾಗದಲ್ಲಿ 4.25ಮೀ. ಅಗಲವಿದ್ದು 24 ಮುಖ್ಯ ನಡುಗಂಬಗಳು ಹಾಗೂ 25 ನೆಪಮಾತ್ರ ನಡುಗಂಬ ಗಳೊಂದಿಗೆ ನಿರ್ಮಿಸಲು ಅಂದಾಜಿನಲ್ಲಿ ವಿನ್ಯಾಸಿಸಿದೆ. ಈ ಬ್ಯಾರೇಜ್‌ನ ಶೇಖರಣಾ ಸಾಮರ್ಥ್ಯ 1.8029 ದಶಲಕ್ಷ ಘನಮೀಟರ್‌ಗಳಾಗಿದ್ದು 240ಹೆ. ಪ್ರದೇಶಕ್ಕೆ ನೀರಾವರಿ ಸೌಲಭ್ಯ ಕಲ್ಪಿಸಲು ಉದ್ದೇಶಿಸಿದೆ. ಈ ಯೋಜನೆಯ ಲಾಭ ವೆಚ್ಚದ ಅನುಪಾತವು ಶೇ. 10ರ ದರದಲ್ಲಿ 1.38 ಆಗಿದ್ದು ಆರ್ಥಿಕವಾಗಿ ಶಕ್ಯವಾಗಿರುತ್ತದೆ.

2011–12ನೇ ಸಾಲಿನ ಮುಂದುವರೆದ ಕಾಮಗಾರಿಗಳ ಅನುಬಂಧ–ಇ ನಲ್ಲಿ ಲೆಕ್ಕಶೀರ್ಷಿಕೆ "4702–00–10–5–01–139 ಆಣೆಕಟ್ಟು ಮತ್ತು ಪಿಕಪ್‌ಗಳ ನಿರ್ಮಾಣ–ಪ್ರಧಾನ ಕಾಮಗಾರಿಗಳುರಡಿ ರೂ. 540.00 ಲಕ್ಷ ಅಂದಾಜು ಮೊತ್ತ ಹಾಗೂ 183.60 ಲಕ್ಷ ಅನುದಾನದೊಂದಿಗೆ ಈ ಕಾಮಗಾರಿಯನ್ನು ಕೈಗೊಳ್ಳಲು ಅವಕಾಶ ಕಲ್ಪಿಸಲಾಗಿರುತ್ತದೆ.

ಪ್ರಸ್ತಾವನೆಯನ್ನು ಕೂಲಂಕುಷವಾಗಿ ಪರಿಶೀಲಿಸಿ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 51 ಅಪಿಬಂ (ತಾಂತ್ರಿಕ) 2012**

**ಬೆಂಗಳೂರು, ದಿನಾಂಕ : 30ನೇ ಮಾರ್ಚ್ 2012.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಹಾವೇರಿ ಜಿಲ್ಲೆ ಹಾನಗಲ್ ತಾಲ್ಲೂಕಿನ ಮಕರವಳ್ಳಿ ಗ್ರಾಮದ ಹತ್ತಿರ ವರದಾ ನದಿಗೆ ಅಡ್ಡಲಾಗಿ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣ ಕಾಮಗಾರಿಯ 2011–12ನೇ ಸಾಲಿಗೆ ಮುಂದುವರೆಸಿರುವ 2010–11ನೇ ಸಾಲಿನ ದರಪಟ್ಟಿಯಂತೆ ತಯಾರಿಸಲಾದ ರೂ.4,99,98,832/–ಗಳ (ನಾಲ್ಕು ಕೋಟಿ ತೊಂಭತ್ತೊಭತ್ತು ಲಕ್ಷ ತೊಂಭತ್ತೆಂಟು ಸಾವಿರದ ಎಂಟುನೂರ ಮೂವತ್ತೆರಡು ಮಾತ್ರ) ಅಂದಾಜು ಪಟ್ಟಿಗೆ ಈ ಕೆಳಕಂಡ ಷರತ್ತಿಗೊಳಪಟ್ಟು ಸರ್ಕಾರವು ಆಡಳಿತಾತ್ಮಕ ಅನುಮೋದನೆ ನೀಡಿದೆ.

1) ಕಾಮಗಾರಿಯ ವೆಚ್ಚವು ಯಾವುದೇ ಕಾರಣಕ್ಕೂ ಅನುಮೋದಿಸಿದ ಟೆಂಡರ್ ಮೊತ್ತಕ್ಕಿಂತ ಹೆಚ್ಚಾಗಬಾರದು ಹಾಗೂ ಕಾಮಗಾರಿಯನ್ನು ಕಾಲಮಿತಿಯೊಳಗೆ ಪೂರ್ಣಗೊಳಿಸತಕ್ಕದ್ದು.
2) ಒಂದುವೇಳೆ ಸ್ಥಳ ಪರಿಸ್ಥಿತಿಗೆ ಅನುಗುಣವಾಗಿ ಹೆಚ್ಚಳ ನಿರೀಕ್ಷಿಸಿದಲ್ಲಿ ತಕ್ಷಣವೇ ಸಕ್ಷಮ ಪ್ರಾಧಿಕಾರದಿಂದ ಅನುಮೋದನೆ ಪಡೆದು ಕಾಮಗಾರಿಯನ್ನು ಪೂರ್ಣಗೊಳಿಸತಕ್ಕದ್ದು.
3) ಕಾಮಗಾರಿ ಪ್ರಾರಂಭಿಸುವ ಮುನ್ನ ವಿನ್ಯಾಸ ಬದಲಾವಣೆಯಿಂದಾಗಿ ಅಥವಾ ಬೇರೆ ಕಾರಣದಿಂದ ಅನುಮೋದಿಸಿದ ಅಂದಾಜು ಮೊತ್ತ ಹೆಚ್ಚಾಗುವ ಸಂಭವ ಇದ್ದಲ್ಲಿ, ತಕ್ಷಣ ಪರಿಷ್ಕೃತ ಅಂದಾಜಿಗೆ ಸಕ್ಷಮ ಪ್ರಾಧಿಕಾರದಿಂದ ಅನುಮೋದನೆ ಪಡೆದು ನಂತರ ಕಾಮಗಾರಿಯನ್ನು ಪ್ರಾರಂಭಿಸುವುದು.
4) ಕಾಮಗಾರಿಯ ಅಂದಾಜು ಪಟ್ಟಿಗೆ ತಾಂತ್ರಿಕ ಮೌಲ್ಯ ನಿರ್ಣಯ ಸಮಿತಿ/ತಾಂತ್ರಿಕ ಸಮಿತಿಯ ತೀರುವಳಿ ಪಡೆಯುವುದು.
5) ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮ 1999ರ ಅನುಸಾರ ಟೆಂಡರ್ ಕರೆದು ತೆಗೆದುಕೊಳ್ಳತಕ್ಕದ್ದು.
6) ಇ.ಐ.ಆರ್.ಎಲ್/ವರ್ಕ್‌ಸ್ಲಿಪ್‌ಗಳನ್ನು ಸಲ್ಲಿಸಬೇಕಾದಲ್ಲಿ ತಕ್ಷಣವೇ ಸಲ್ಲಿಸತಕ್ಕದ್ದು.
7) ತಾಂತ್ರಿಕ ಮಂಜೂರಾತಿಯನ್ನು ನೀಡುವ ಮೊದಲು ಅಂದಾಜನ್ನು ಮತ್ತೊಮ್ಮೆ ವಿವರವಾಗಿ ಪರಿಶೀಲಿಸುವುದು.
8) ಈ ಯೋಜನೆಗೆ ನೀರು ಬಳಕೆದಾರರ ಸಂಘನ್ನು ಸೃಜಿಸುವುದು.

ಈ ಆದೇಶವನ್ನು ಸರ್ಕಾರದ ಆದೇಶ ಸಂಖ್ಯೆ: ಎಫ್‌ಡಿ. 1 ಟಿ.ಎಫ್.ಪಿ 2008 ದಿನಾಂಕ: 16–05–2008ರಲ್ಲಿ ಇಲಾಖಾ ಕಾರ್ಯದರ್ಶಿಗಳಿಗೆ ಪ್ರತ್ಯಾಯೋಜಿಸಿರುವ ಅಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ರುದ್ರಮೂರ್ತಿ**

ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,

ಪಿ.ಆರ್. 1108 ಜಲ ಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ :** ಬಿಜಾಪುರ ಜಿಲ್ಲೆ ಇಂಡಿ ತಾಲ್ಲೂಕಿನ ಬೆನಕನಹಳ್ಳಿ ಗ್ರಾಮದ ಕೂಡಲ ಹತ್ತಿರ ದೊಡ್ಡ ಹಳ್ಳಕ್ಕೆ ಅಡ್ಡಲಾಗಿ ಬ್ಯಾರೇಜ್ ನಿರ್ಮಾಣ ಕಾಮಗಾರಿಯ ಟೆಂಡರ್ ಅನುಮೋದಿಸುವ ಬಗ್ಗೆ.

**ಓದಲಾಗಿದೆ :**

1. ಸರ್ಕಾರದ ಆದೇಶ ಸಂಖ್ಯೆ: ಸನೀಇ 03 ನಯೋಕಾ 2011, ದಿನಾಂಕ: 29–12–2011.
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರರವರ ಪತ್ರದ ಕ್ರಮಾಂಕ: ಮುಇಂ/ಸನೀ(ಉ)ವಲಯ/ಬಿಜೆಪಿ/ಪಿಬಿ–9/ಬೆನಕನಹಳ್ಳಿಯ ಕೂಡಲ ಬ್ಯಾರೇಜ್ 2011–12/1453, ದಿನಾಂಕ: 14–03–2012.

**ಪ್ರಸ್ತಾವನೆ:–**

ಬಿಜಾಪುರ ಜಿಲ್ಲೆ ಇಂಡಿ ತಾಲ್ಲೂಕಿನ ಬೆನಕನಹಳ್ಳಿ ಗ್ರಾಮದ ಕೂಡಲ ಹತ್ತಿರ ದೊಡ್ಡ ಹಳ್ಳಕ್ಕೆ ಅಡ್ಡಲಾಗಿ ಬ್ಯಾರೇಜ್ ನಿರ್ಮಾಣ ಕಾಮಗಾರಿ ಅಂದಾಜಿಗೆ ಉಲ್ಲೇಖ (1) ರಲ್ಲಿ ನಮೂದಿಸಿರುವ ಸರ್ಕಾರದ ಆದೇಶದಲ್ಲಿ ಆಡಳಿತಾತ್ಮಕ ಅನುಮೋದನೆ ನೀಡಲಾಗಿದ್ದು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರು ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಬಿಜಾಪುರ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್‌ನ ಪ್ರಕಟಣೆಯನ್ನು ಈ ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ರಾಜ್ಯ ಟೆಂಡರ್ ಬುಲೆಟಿನ್ | 24–01–2012 |
| ಪ್ರಜಾವಾಣಿ ದಿನ ಪತ್ರಿಕೆ | 24–01–2012 |
| ಟೈಮ್ಸ್ ಆಫ್ ಇಂಡಿಯಾ ಆಂಗ್ಲ ದಿನ ಪತ್ರಿಕೆ | 24–01–2012 |

ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಇಬ್ಬರು ಗುತ್ತಿಗೆದಾರರು ಮಾತ್ರ ಭಾಗವಹಿಸಿದ್ದು ಈ ಪೈಕಿ ಒಬ್ಬರು ಗುತ್ತಿಗೆದಾರರು ಮಾತ್ರ ಅರ್ಹತೆ ಹೊಂದಿದ್ದು ಇವರ ಆರ್ಥಿಕ ಬಿಡ್‌ಅನ್ನು ದಿನಾಂಕ 10–03–2012 ರಂದು ತೆರೆಯಲಾಗಿದ್ದು ವಿವರಗಳು ಕೆಳಕಂಡಂತಿವೆ.

| | | | |
|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 3,23,32,288/– |
| ಪ್ರಸಕ್ತ ಸಾಲಿನ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 3,24,41, 175/– |
| ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ | ಹಾಗೂ ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| ಜಿ.ಮಸ್ತಾನಯ್ಯ, ಒಂದನೇ ದರ್ಜೆ ಗುತ್ತಿಗೆದಾರರು | 3,45,85,730/– | 6.96 ಹೆಚ್ಚು | 6.61 ಹೆಚ್ಚು |

ಮೇಲ್ಕಂಡಂತೆ ಶ್ರೀ ಜಿ. ಮಸ್ತಾನಯ್ಯ, ಒಂದನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿರುವ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 6.61ರಷ್ಟು ಹೆಚ್ಚಾಗಿದ್ದು, ಸದರಿಯವರ ಟೆಂಡರನ್ನು ಸಂಧಾನದ ಮೂಲಕ ಅಂಗೀಕರಿಸಲು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ ಓದಲಾದ ಪತ್ರದಲ್ಲಿ ಶಿಫಾರಸ್ಸು ಮಾಡಿರುತ್ತಾರೆ.

ಈ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 3,24,41,175/– ಗಳ ಮೇಲೆ ಶೇ. 6.60ರಷ್ಟು ಹೆಚ್ಚಿನ ದರದಲ್ಲಿ ಅಂದರೆ ರೂ. 3,45,82,293/–ಗಳಿಗೆ ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 42 ಅಪಿಬಂ 2012 (ತಾಂತ್ರಿಕ)**

**ಬೆಂಗಳೂರು, ದಿನಾಂಕ : 29ನೇ ಮಾರ್ಚ್ 2012.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬಿಜಾಪುರ ಜಿಲ್ಲೆ ಇಂಡಿ ತಾಲ್ಲೂಕಿನ ಬೆನಕನಹಳ್ಳಿ ಗ್ರಾಮದ ಕೂಡಲ ಹತ್ತಿರ ದೊಡ್ಡ ಹಳ್ಳಕ್ಕೆ ಅಡ್ಡಲಾಗಿ ಬ್ಯಾರೇಜ್ ನಿರ್ಮಾಣ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಡಲಾದ ಮೊತ್ತ ರೂ. 3,24,41,175/–ಗಳ ಮೇಲೆ ಶೇ. 6.60ರಷ್ಟು ಹೆಚ್ಚಿನ ದರದಲ್ಲಿ ಅಂದರೆ ರೂ. 3,45,82,293/–ಗಳಿಗೆ (ರೂ. ಮೂರು ಕೋಟಿ ನಲವತ್ತೈದು ಲಕ್ಷ ಎಂಭತ್ತೆರಡು ಸಾವಿರದ ಇನ್ನೂರ ತೊಂಭತ್ತಮೂರು ಮಾತ್ರ) ಗಳಿಗೆ ಶ್ರೀ ಜಿ. ಮಸ್ತಾನಯ್ಯ, ಒಂದನೇ ದರ್ಜೆ ಗುತ್ತಿಗೆದಾರರುರವರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗದಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ 20–01–2003ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ರುದ್ರಮೂರ್ತಿ**

ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,

ಪಿ.ಆರ್. 1109 ಜಲ ಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

## PERSONNEL AND ADMINISTRATIVE REFORMS SECRETARIAT

## CORRIGENDUM

No. DPAR 31 SeVuNya 2011, Bangalore, Dated: 4th April 2012.

The words "Government Order No. DPAR 31 SeVuNya 2011 Bangalore Dated 21-03-2011" appearing after preamble portion, in Government Order No. DPAR 31 SeVuNya 2011 Bangalore Dated: 21-03-2011 may be read as **"Government Order No. DPAR 31 SeVuNya 2011 Bangalore Dated 21-03-2012".**

By Order and in the name of the Governor of Karnataka,

**A.R. VIJAYANANDA SHARMA**

Under Secretary to Government

P.R.1110 D.P.A.R. (Services-3)

## ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಸಚಿವಾಲಯ

**ವಿಷಯ:** ನೆಮ್ಮದಿ ಗ್ರಾಮೀಣ ಟೆಲಿಸೆಂಟರ್‌ಗಳ ಮತ್ತು ತಾಲ್ಲೂಕು ಹಿಂಬದಿ ಕಛೇರಿಗಳ ನಿರ್ವಹಣೆಯನ್ನು ಪರ್ಯಾಯ ವ್ಯವಸ್ಥೆ ಮಾಡುವವರೆಗೆ, ಮಧ್ಯಂತರ ವ್ಯವಸ್ಥೆಯನ್ನಾಗಿ ದಿನಾಂಕ: 01–02–2012 ರ ನಂತರವೂ ಮುಂದುವರೆಸುವ ಬಗ್ಗೆ.

**ಓದಲಾಗಿದೆ:**
1) ದಿನಾಂಕ: 17–12–2005ರ ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 82 ವಿಮಾಆ 2005.
2) ದಿನಾಂಕ: 22–04–2006ರ ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 82 ವಿಮಾಆ 2005.
3) ದಿನಾಂಕ: 22–04–2006ರ ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 82 ವಿಮಾಆ 2005 (ಅದೇ ದಿನಾಂಕ ಮತ್ತು ಸಂಖ್ಯೆಯ ಎರಡನೇ ಆದೇಶ).
4) ದಿನಾಂಕ: 04–09–2006ರ ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 82 ವಿಮಾಆ 2005.
5) ದಿನಾಂಕ: 04–09–2006ರ ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 82 ವಿಮಾಆ 2005. (ಅದೇ ದಿನಾಂಕ ಮತ್ತು ಸಂಖ್ಯೆಯ ಎರಡನೇ ಆದೇಶ).
6) ದಿನಾಂಕ: 27–07–2007ರ ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 01 ಆರ್‌ಐಟಿ 2007.
7) ದಿನಾಂಕ: 19–09–2011ರ ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 2 ಆರ್‌ಐಟಿ 2011.
8) ದಿನಾಂಕ: 13–12–2011ರಂದು ಮುಖ್ಯ ಕಾರ್ಯದರ್ಶಿಯವರ ಅಧ್ಯಕ್ಷತೆಯಲ್ಲಿ ನಡೆದ ಸಭೆಯ ನಡವಳಿ.
9) ದಿನಾಂಕ: 07–02–2012ರ ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 1 ಪಿಆರ್‌ಜೆ 2012 (ಭಾಗ–2)

**ಪ್ರಸ್ತಾವನೆ:**

1. ನೆಮ್ಮದಿ ಯೋಜನೆ ನಿರ್ವಹಣೆಯ ಉಸ್ತುವಾರಿ ಮಾಡುವ ಸಲುವಾಗಿ ಅಪರ ಮುಖ್ಯ ಕಾರ್ಯದರ್ಶಿಯವರ ಅಧ್ಯಕ್ಷತೆಯಲ್ಲಿ ಮೇಲೆ (1)ರಲ್ಲಿ ಓದಲಾದ ದಿನಾಂಕ: 17–12–2005ರ ಸರ್ಕಾರಿ ಆದೇಶದನ್ವಯ ಸಮಿತಿಯನ್ನು ರಚಿಸಲಾಯಿತು. ನೆಮ್ಮದಿ ಯೋಜನೆಯಡಿ ಹೋಬಳಿ ಮಟ್ಟದಲ್ಲಿ 800 ಟೆಲಿಸೆಂಟರ್‌ಗಳನ್ನು ಸ್ಥಾಪಿಸುವ ಸಲುವಾಗಿ ಕರೆದ ಟೆಂಡರ್‌ಗಳ ಪರಿಶೀಲನೆಗಾಗಿ ಟೆಂಡರ್ ಪರಿಶೀಲನಾ ಸಮಿತಿಯನ್ನು ಮೇಲೆ (2)ರಲ್ಲಿ ಓದಲಾದ ದಿನಾಂಕ: 22–04–2006ರ ಸರ್ಕಾರಿ ಆದೇಶದನ್ವಯ ರಚಿಸಲಾಯಿತು. ಮೇಲೆ (3)ರಲ್ಲಿ ಓದಲಾದ ದಿನಾಂಕ: 22—04–2006ರ ಸರ್ಕಾರಿ ಆದೇಶದನ್ವಯ ಸದರಿ ಟೆಂಡರ್‌ಗಳಿಗೆ ಸಂಬಂಧಿಸಿದಂತೆ ಟೆಂಡರ್ ಅಂಗೀಕರಿಸುವ ಸಮಿತಿಯನ್ನು ರಚಿಸಲಾಯಿತು. ಅದಾದ ನಂತರ. ಉತ್ತರ ಕರ್ನಾಟಕದ 14 ಜಿಲ್ಲೆಗಳಲ್ಲಿ 400 ಟೆಲಿಸೆಂಟರ್, 86 ತಾಲ್ಲೂಕು ಹಿಂಬದಿ (ಆರ್‌ಡಿಎಸ್) ಕಚೇರಿಗಳನ್ನು ಸ್ಥಾಪಿಸಲು ಮತ್ತು ನಿರ್ವಹಿಸಲು ಮೇಲೆ (4)ರಲ್ಲಿ ಓದಲಾದ ದಿನಾಂಕ: 04–09–2006ರ ಸರ್ಕಾರಿ ಆದೇಶದನ್ವಯ ನೆಮ್ಮದಿ ಯೋಜನೆಯ ಯಶಸ್ವಿ ಬಿಡ್ಡುದಾರರು (ಖಾಸಗಿ ಪಾಲುದಾರರು) ಅದ ಮೆ. 3ಐ ಇನ್ಫೋಟೆಕ್ ಲಿ. ನೇತೃತ್ವದ ಸಮೂಹದೊಂದಿಗೆ ಒಪ್ಪಂದವನ್ನು ಮಾಡಿಕೊಳ್ಳಲು ಮಂಜೂರಾತಿಯನ್ನು ನೀಡಲಾಯಿತು. ಅದೇ ರೀತಿ ದಕ್ಷಿಣ ಕರ್ನಾಟಕದ 13 ಜಿಲ್ಲೆಗಳಲ್ಲಿ 400 ಟೆಲಿಸೆಂಟರ್, 78 ತಾಲ್ಲೂಕು ಹಿಂಬದಿ (ಆರ್‌ಡಿಎಸ್) ಕಛೇರಿಗಳನ್ನು ಸ್ಥಾಪಿಸಲು

ಮತ್ತು ನಿರ್ವಹಿಸಲು ಮೇಲೆ (5)ರಲ್ಲಿ ಓದಲಾದ ದಿನಾಂಕ: 04-09-2006ರ ಸರ್ಕಾರಿ ಆದೇಶದನ್ವಯ ಸದರಿ ಸಮೂಹದೊಂದಿಗೆ ಒಪ್ಪಂದವನ್ನು ಮಾಡಿಕೊಳ್ಳಲು ಮಂಜೂರಾತಿಯನ್ನು ನೀಡಲಾಯಿತು. ನೆಮ್ಮದಿ ಯೋಜನೆಯ ಪರಿಣಾಮಕಾರಿ ನಿರ್ವಹಣೆಗಾಗಿ ಮೇಲೆ (6)ರಲ್ಲಿ ಓದಲಾದ ದಿನಾಂಕ: 27-07-2007ರ ಸರ್ಕಾರಿ ಆದೇಶದನ್ವಯ ಜಿಲ್ಲಾಧಿಕಾರಿಯವರ ಅಧ್ಯಕ್ಷತೆಯಲ್ಲಿ ಜಿಲ್ಲಾ ಮಟ್ಟದ ಸಮನ್ವಯ ಸಮಿತಿಯನ್ನು ರಚಿಸಲು ಮಂಜೂರಾತಿಯನ್ನು ನೀಡಲಾಗಿದೆ. ನಿಷ್ಕ್ರಮಣ ನಿರ್ವಹಣಾ ಯೋಜನೆ (exit management plan) ಯ ಮೌಲ್ಯಮಾಪನ ಮಾಡಿ ಅದನ್ನು ಅಂತಿಮಗೊಳಿಸಲು ಹಾಗೂ ಕೆಲವು ಬಾಕಿಯಿರಬಹುದಾದ ವಿಷಯಗಳನ್ನು ಬಗೆಹರಿಸಲು ನೆಮ್ಮದಿ ಯೋಜನೆಗೆ ಸಂಬಂಧಿಸಿದವರನ್ನು ಒಳಗೊಂಡ ಸಮಿತಿಯನ್ನು ಮೇಲೆ (7)ರಲ್ಲಿ ಓದಲಾದ ದಿನಾಂಕ: 19-09-2011ರ ಅದೇಶದನ್ವಯ ರಚಿಸಲಾಗಿದೆ.

2. ನೆಮ್ಮದಿ ಯೋಜನೆಯ ಖಾಸಗಿ ಪಾಲುದಾರರೊಂದಿಗೆ ಮಾಡಲಾದ ಒಪ್ಪಂದದ ಅವಧಿ ದಿನಾಂಕ: 01-09-2006ರಂದು ಪ್ರಾರಂಭವಾಗಿ, ದಿನಾಂಕ: 31-01-2012ರಂದು ಮುಕ್ತಾಯವಾಗಿದ್ದು, ಇದರಲ್ಲಿ ನಾಲ್ಕು ತಿಂಗಳ ನಿಷ್ಕ್ರಮಣ ನಿರ್ವಹಣಾ ಅವಧಿಯು (exit management period) ಸಹ ಒಳಗೊಂಡಿರುತ್ತದೆ. ಆದುದರಿಂದ. ನೆಮ್ಮದಿ ಗ್ರಾಮೀಣ ಟೆಲಿಸೆಂಟರ್‌ಗಳ ಮತ್ತು ತಾಲ್ಲೂಕು ಹಿಂಬದಿ ಕಚೇರಿಗಳ ನಿರ್ವಹಣೆಯನ್ನು ಪರ್ಯಾಯ ವ್ಯವಸ್ಥೆ ಮಾಡುವವರಗೆ, ಮಧ್ಯಂತರ ವ್ಯವಸ್ಥೆಯನ್ನಾಗಿ, ದಿನಾಂಕ: 01-02-2012ರ ನಂತರವೂ ಮುಂದುವರೆಸುವ ಅಗತ್ಯತೆಯ ಬಗ್ಗೆ ಸರ್ಕಾರ ಪರಿಶೀಲಿಸಿದೆ. ಈ ಕೆಳಕಂಡ ಕಾರಣಗಳಿಗಾಗಿ ನೆಮ್ಮದಿ ಗ್ರಾಮೀಣ ಟೆಲಿಸೆಂಟರ್‌ಗಳ ಮತ್ತು ತಾಲ್ಲೂಕು ಹಿಂಬದಿ ಕಛೇರಿಗಳ ನಿರ್ವಹಣೆಯನ್ನು ಮುಂದುವರೆಸುವುದು ಅಗತ್ಯವೆಂದು ಸರ್ಕಾರ ಭಾವಿಸಿದೆ:-

1. ಗ್ರಾಮೀಣ ಪ್ರದೇಶದ ನಿವಾಸಿಗಳಿಗೆ ವಿವಿಧ ಸೇವೆಗಳನ್ನು ಒದಗಿಸುತ್ತಿರುವ ನೆಮ್ಮದಿ ಕೇಂದ್ರಗಳ ಕಾರ್ಯನಿರ್ವಹಣೆಯನ್ನು ನಿಲ್ಲಿಸದೇ ಮುಂದುವರೆಸಬೇಕೆಂದು ದಿನಾಂಕ: 23-08-2011ರಂದು ನೆಮ್ಮದಿ ಕೇಂದ್ರಗಳ ನಿರ್ವಹಣೆಯ ಕುರಿತಂತೆ ಮಾನ್ಯ ಮುಖ್ಯಮಂತ್ರಿಯವರ ಅಧ್ಯಕ್ಷತೆಯಲ್ಲಿ ನಡೆದ ಸಭೆಯಲ್ಲಿ ನಿರ್ಣಯಿಸಲಾಗಿದೆ.
2. ಏಪ್ರಿಲ್, ಮೇ, ಜೂನ್, ಜುಲೈ ಮತ್ತು ಆಗಸ್ಟ್ ತಿಂಗಳುಗಳಲ್ಲಿ ಪಹಣಿ ಪತ್ರ, ಜಾತಿ ಮತ್ತು ವರಮಾನ ಪ್ರಮಾಣ ಪತ್ರಗಳ ಬೇಡಿಕೆ ಅತೀ ಹೆಚ್ಚಿರುತ್ತದೆ. ಸರ್ಕಾರದ ವಿವಿಧ ಯೋಜನೆಗಳ ಅಡಿಯಲ್ಲಿ ಲಭ್ಯವಿರುವ ಸೌಲಭ್ಯಗಳನ್ನು ಪಡೆಯುವ ಸಲುವಾಗಿ ಹಾಗೂ ಶಾಲಾ ಕಾಲೇಜು ದಾಖಲೆಗಾಗಿ ವಿದ್ಯಾರ್ಥಿಗಳು ಜಾತಿ ಮತ್ತು ವರಮಾನ ಪ್ರಮಾಣ ಪತ್ರಗಳನ್ನು ಪಡೆಯಬೇಕಾಗುತ್ತದೆ.
3. ಸರ್ಕಾರ ಘೋಷಿಸುವ ವಿವಿಧ ಯೋಜನೆಗಳ ಅಡಿಯಲ್ಲಿ ಲಭ್ಯವಾಗುವ ಸೌಲಭ್ಯಗಳನ್ನು ಪಡೆಯುವ ಸಲುವಾಗಿ ರೈತರು ಪಹಣಿ ಪತ್ರಗಳನ್ನು ಪಡೆಯಬೇಕಾಗುತ್ತದೆ.
4. ಮೇಲಿನ ಅಂಶ (2) ಮತ್ತು (3)ರ ಹಿನ್ನೆಲೆಯಲ್ಲಿ, ನೆಮ್ಮದಿ ಯೋಜನೆಯ ಮೂಲಕ ನೀಡುವ ಸೇವೆಗಳನ್ನು ನಿಲ್ಲಿಸಿದಲ್ಲಿ, ಇದರಿಂದಾಗಿ ಗ್ರಾಮೀಣ ಪ್ರದೇಶದ ನಿವಾಸಿಗಳಿಗೆ ವಿಶೇಷವಾಗಿ ರೈತರಿಗೆ ಮತ್ತು ವಿದ್ಯಾರ್ಥಿಗಳಿಗೆ ತೊಂದರೆಯಾಗುತ್ತದೆ.
5. ಮೇಲೆ ಹೇಳಿದಂತೆ, ನೆಮ್ಮದಿ ಯೋಜನೆಯ ಖಾಸಗಿ ಪಾಲುದಾರರೊಂದಿಗೆ ಮಾಡಲಾದ ಒಪ್ಪಂದದ ಅವಧಿ ದಿನಾಂಕ: 01-09-2006ರ ರಂದು ಪ್ರಾರಂಭವಾಗಿ, ದಿನಾಂಕ: 31-01-2012 ರಂದು ಮುಕ್ತಾಯವಾಗಿದ್ದು, ಇದರಲ್ಲಿ ನಾಲ್ಕು ತಿಂಗಳ ನಿಷ್ಕ್ರಮಣ ನಿರ್ವಹಣಾ ಅವಧಿಯು (exit management period) ಸಹ ಒಳಗೊಂಡಿರುತ್ತದೆ. ಹೊಸ ವ್ಯವಸ್ಥೆಯನ್ನು ಜಾರಿಗೆ ತರುವ ಪ್ರಕ್ರಿಯೆ ಜಾರಿಯಲ್ಲಿದೆ. ಆ ಪ್ರಕ್ರಿಯೆಯನ್ನು ಪೂರ್ಣಗೊಳಿಸಲು ಸಾಕಷ್ಟು ಕಾಲಾವಕಾಶ ಬೇಕಾಗುತ್ತದೆ. ಅದು ಪೂರ್ಣಗೊಳ್ಳುವವರೆಗೆ ಒಂದು ಪರ್ಯಾಯ/ತಾತ್ಕಾಲಿಕ ವ್ಯವಸ್ಥೆಯನ್ನು ಕೂಡಲೇ ಜಾರಿಗೆ ತರುವುದು ಅಗತ್ಯವಾಗಿದೆ. ಮೇಲೆ (9)ರಲ್ಲಿ ಓದಲಾದ ದಿನಾಂಕ: 07-02-2012ರ ಸರ್ಕಾರಿ ಆದೇಶದನ್ವಯ. ನೆಮ್ಮದಿ ಗ್ರಾಮೀಣ ಟೆಲಿಸೆಂಟರ್‌ಗಳ ಮತ್ತು ತಾಲ್ಲೂಕು ಹಿಂಬದಿ ಕಛೇರಿಗಳ ನಿರ್ವಹಣೆಯನ್ನು ಹೊಸ (ಪರ್ಯಾಯ) ವ್ಯವಸ್ಥೆ ಮಾಡುವವರೆಗೆ, ಮಧ್ಯಂತರ ವ್ಯವಸ್ಥೆಯನ್ನಾಗಿ, ದಿನಾಂಕ: 01-02-2012 ರಿಂದ ಜಾರಿಗೆ ಬರುವಂತೆ ಮೆ. ಕರ್ನಾಟಕ ರಾಜ್ಯ ವಿದ್ಯುನ್ಮಾನ ಅಭಿವೃದ್ಧಿ ನಿಗಮ ನಿಯಮಿತಕ್ಕೆ ವಹಿಸತಕ್ಕದೆಂದು ಆದೇಶಿಸಲಾಗಿದೆ. ತದನಂತರ. ಈ ವಿಷಯವನ್ನು ಸರ್ಕಾರ ಈ ಕೆಳಕಂಡ ಕಾರಣಗಳಿಗಾಗಿ ಸಮಗ್ರವಾಗಿ ಪುನರ್ ಪರಿಶೀಲಿಸಿದೆ:-

(ಅ) ಈಗಾಗಲೇ ಹೇಳಿದಂತೆ, ನೆಮ್ಮದಿ ಯೋಜನೆಯ ಮುಖ್ಯ ಪಾಲುದಾರರಾಗಿದ್ದ ಮೆ. 3ಐ ಇನ್‌ಫೋಟೆಕ್ ಸಂಸ್ಥೆಯು, ದಿನಾಂಕ: 29-08-2011ರ ತನ್ನ ಪತ್ರದನ್ವಯ ದಿನಾಂಕ 31-01-2012 ರಿಂದ ತಾವು ನೀಡುತ್ತಿರುವ ಸೇವೆಯನ್ನು ನಿಲ್ಲಿಸುವುದಾಗಿಯೂ ಮತ್ತು ನಿಷ್ಕ್ರಮಣಾ ನಿರ್ವಹಣಾ ಅವಧಿಯ ಮುಕ್ತಾಯದ ನಂತರ ಟೆಲಿಸೆಂಟರ್‌ಗಳ ನಿರ್ವಹಣೆಯನ್ನು ಮುಂದುವರೆಸಲು ಇಚ್ಛಿಸುವುದಿಲ್ಲ ಎಂದು ತಿಳಿಸಿರುವ ಕಾರಣ ಮತ್ತು ಸಾರ್ವಜನಿಕರಿಗೆ ಅಡೆತಡೆಯಿಲ್ಲದೆ ಸೇವೆಗಳನ್ನು ನೆಮ್ಮದಿ ಕೇಂದ್ರಗಳ ಮೂಲಕ ನೀಡಲು ಅನುವಾಗಲು ಮಧ್ಯಂತರ ವ್ಯವಸ್ಥೆಯ ಅಗತ್ಯತೆ ಮತ್ತು

(ಆ) ಮೇಲಿನ ಉಪ ಕಂಡಿಕೆ (5)ರಲ್ಲಿ ಉಲ್ಲೇಖಿಸಿದ ಮೆ. ಕರ್ನಾಟಕ ರಾಜ್ಯ ವಿದ್ಯುನ್ಮಾನ ಅಭಿವೃದ್ಧಿ ನಿಗಮ ನಿಯಮಿತವು ಸದರಿ ಸಮೂಹದ ಪಾಲುದಾರರಾದ ಮೆ. ಮೈ ಷೋರ್ ಐಟಿ ಸಲ್ಯೂಷನ್ಸ್ ಪ್ರೈವೇಟ್ ಲಿಮಿಟೆಡ್ ರವರಗೆ ನೆಮ್ಮದಿ ಕೇಂದ್ರಗಳ ನಿರ್ವಹಣೆಯನ್ನು ವಹಿಸಲು ಉದ್ದೇಶಿಸಿದ್ದು. ಆ ಕಾರ್ಯವನ್ನು ಪರೋಕ್ಷವಾಗಿ ಮೆ. ಕರ್ನಾಟಕ ರಾಜ್ಯ ವಿದ್ಯುನ್ಮಾನ ಅಭಿವೃದ್ಧಿ ನಿಗಮ ನಿಯಮಿತದ ಮೂಲಕ ವಹಿಸುವ ಬದಲು, ನೇರವಾಗಿ ಅದನ್ನು ಮೆ. ಮೈ ಷೋರ್ ಐಟಿ ಸಲ್ಯೂಷನ್ಸ್ ಪ್ರೈವೇಟ್ ಲಿಮಿಟೆಡ್ ರವರಿಗೆ ವಹಿಸುವುದು ಸೂಕ್ತವಾಗುವುದೆಂಬ ಕಾರಣ.

3. ಮೇಲೆ ವಿವರಿಸಿದ ಹಿನ್ನೆಲೆಯಲ್ಲಿ, ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 01 ಯೋಜನೆ 2012, ದಿನಾಂಕ 20-03-2012**

ಪ್ರಸ್ತಾವನೆಯಲ್ಲಿ ವಿವರಿಸಿದ ಹಿನ್ನೆಲೆಯಲ್ಲಿ, ಸರ್ಕಾರವು ಈ ಕೆಳಕಂಡಂತೆ ಈ ಮೂಲಕ ಆದೇಶಿಸಿದೆ.

(ಅ) ದಿನಾಂಕ 01–02–2012 ರಿಂದ ನೆಮ್ಮದಿ ಕೇಂದ್ರಗಳ ಮತ್ತು ತಾಲ್ಲೂಕು ಹಿಂಬದಿ ಕಛೇರಿಗಳ ಕಾರ್ಯ ನಿರ್ವಹಣೆಯನ್ನು ಮಧ್ಯಂತರ ವ್ಯವಸ್ಥೆಯನ್ನಾಗಿ. ಒಂದು ವರ್ಷದ ಅವಧಿಗೆ ಅಥವಾ ಪರ್ಯಾಯ ವ್ಯವಸ್ಥೆ ಜಾರಿಯಾಗುವವರೆವಿಗೆ. ಇವುಗಳಲ್ಲಿ ಯಾವುದು ಮೊದಲೋ ಅಲ್ಲಿಯವರೆವಿಗೆ ಮೆ. ಮೈ ಷೋರ್ ಐಟಿ ಸಲ್ಯೂಷನ್ಸ್ ಪ್ರೈವೇಟ್ ಲಿಮಿಟೆಡ್ ಇವರಿಗೆ ವಹಿಸತಕ್ಕದ್ದು.

(ಆ) ದಿನಾಂಕ: 01–02–2012 ರಿಂದ ನೆಮ್ಮದಿ ಕೇಂದ್ರಗಳ ಮತ್ತು ತಾಲ್ಲೂಕು ಹಿಂಬದಿ ಕಛೇರಿಗಳ ಕಾರ್ಯ ನಿರ್ವಹಣೆಯನ್ನು ಮಧ್ಯಂತರ ವ್ಯವಸ್ಥೆಯನ್ನಾಗಿ ಒಂದು ವರ್ಷದ ಅವಧಿಗೆ ಅಥವಾ ಪಯಾರ್ಯ ವ್ಯವಸ್ಥೆ ಜಾರಿಯಾಗುವವರೆವಿಗೆ ಇವುಗಳಲ್ಲಿ ಯಾವುದು ಮೊದಲೋ ಅಲ್ಲಿಯವರೆವಿಗೆ ಮೆ. ಮೈ ಷೋರ್ ಐಟಿ ಸಲ್ಯೂಷನ್ಸ್ ಪ್ರೈವೇಟ್ ಲಿಮಿಟೆಡ್ ಇವರಿಗೆ ನೇರವಾಗಿ ವಹಿಸಲು ಕರ್ನಾಟಕ ಸಾರ್ವಜನಿಕ ಸಂಗ್ರಹಣೆಯಲ್ಲಿ ಪಾರದರ್ಶಕತೆ ಅಧಿನಿಯಮ, 1999ರ ಕಲಂ 4(ಜಿ) ರಡಿ ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ಇ–ಆಡಳಿತ) ಗೆ ವಿನಾಯಿತಿಯನ್ನು ನೀಡತಕ್ಕದ್ದು.

(ಇ) ಪ್ರತಿ ಆರ್‌ಟಿಸಿ ವಿತರಣೆಗೆ ಏಕರೂಪದ ರೂ. 7.50 (ಏಳು ರೂಪಾಯಿ ಐವತ್ತು ಪೈಸೆ) ರ ವ್ಯವಹಾರ ಸೇವಾ ಶುಲ್ಕವನ್ನು ನಿಗದಿಪಡಸತಕ್ಕದ್ದು ಮತ್ತು ಬಾಕಿ ಉಳಿಯುವ ರೂ. 2.50 (ಎರಡು ರೂಪಾಯಿ ಐವತ್ತು ಪೈಸೆ) ನ್ನು ಜಿಲ್ಲಾಧಿಕಾರಿಗಳಿಗೆ ವರ್ಗಾಯಿಸತಕ್ಕದ್ದು.

(ಈ) ಬಿ ಮತ್ತು ಸಿ ವರ್ಗದ ಪ್ರತಿ ಆರ್‌ಡಿಎಸ್ ಪ್ರಮಾಣ ಪತ್ರದ ವಿತರಣೆಗೆ ಏಕರೂಪದ ರೂ. 15.00 (ಹದಿನೈದು ರೂಪಾಯಿ) ರ ವ್ಯವಹಾರ ಸೇವಾ ಶಿಲ್ಕವನ್ನು ನಿಗದಿಪಡಿಸತಕ್ಕದ್ದು ಮತ್ತು 'ಎ' ವರ್ಗದ ಪ್ರತಿ ಪ್ರಮಾಣ ಪತ್ರದ ವಿತರಣೆಗೆ ರೂ. 5.00 (ಐದು ರೂಪಾಯಿ) ನಿಗದಿಪಡಿಸತಕ್ಕದ್ದು.

(ಉ) ಮೋಜಿಣೀ ಸೇವೆಗೆ ಸಂಬಂಧಿಸಿದಂತೆ ಅಪರ ಮುಖ್ಯ ಕಾರ್ಯದರ್ಶಿಯವರ ಅಧ್ಯಕ್ಷತೆಯಲ್ಲಿರುವ ರಾಜ್ಯ ಮಟ್ಟದ ಸಮಿತಿಯು ನಿಗದಿಪಡಿಸುವ ವ್ಯವಹಾರ ಸೇವಾ ಶುಲ್ಕದ ರಚನೆ (transaction service fee structure) ಯನ್ನು ಅಳವಡಿಸತಕ್ಕದ್ದು ಮತ್ತು

(ಊ) ಮೇಲೆ (8)ರಲ್ಲಿ ಓದಲಾದ, ದಿನಾಂಕ: 13–12–2011ರಂದು ಮುಖ್ಯ ಕಾರ್ಯದರ್ಶಿಯವರ ಅಧ್ಯಕ್ಷತೆಯಲ್ಲಿ ನಡೆದ ಸಭೆಯ ನಡವಳಿಯಂತೆ, ಕಾರ್ಯಸಾಧ್ಯತೆಯ (viability) ಅಂಶಗಳ ಹಿನ್ನೆಲೆಯಲ್ಲಿ, ಗ್ರಾಮ ಪಂಚಾಯಿತಿಗಳಲ್ಲಿ ಸಾಮಾನ್ಯ ಸೇವಾ ಕೇಂದ್ರಗಳನ್ನು ರಚಿಸುವ ಕೇಂದ್ರ ಸರ್ಕಾರದ ಯೋಜನೆಯನ್ನು ಕರ್ನಾಟಕ ರಾಜ್ಯದಲ್ಲಿ ಜಾರಿಗೊಳಿಸುವುದನ್ನು ಈ ಹಂತದಲ್ಲಿ ಕೈಬಿಡಲು ಮತ್ತು ಕರ್ನಾಟಕ ರಾಜ್ಯದಲ್ಲಿ ಸದರಿ ಸಾಮಾನ್ಯ ಸೇವಾ ಕೇಂದ್ರಗಳನ್ನು ಸ್ಥಾಪಿಸಲು ಮತ್ತು ನಿರ್ವಹಿಸಲು ಸಂಸ್ಥೆಗಳನ್ನು ಆಯ್ಕೆಗೆ ಸಂಬಂಧಿಸಿದ ಸಂಪೂರ್ಣ ಪ್ರಕ್ರಿಯೆಯನ್ನು ರದ್ದುಪಡಿಸತಕ್ಕದ್ದು.

5. ಈ ಆದೇಶದ ಹಿನ್ನೆಲೆಯಲ್ಲಿ ಮೇಲೆ (9) ರಲ್ಲಿ ಓದಲಾದ ದಿನಾಂಕ: 07–02–2012ರ ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 1 ಯೋಜನೆ 2012 (ಭಾಗ–2) ವನ್ನು ಈ ಮೂಲಕ ರದ್ದುಪಡಿಸಲಾಗಿದೆ.

6. ಆರ್ಥಿಕ ಇಲಾಖೆ ದಿನಾಂಕ: 15–02–2012ರ ಟಿಪ್ಪಣಿ ಸಂಖ್ಯೆ: ಆಇ /180/ವೆಚ್ಚ–7/2012ರನ್ವಯ ನೀಡಿದ ಸಹಮತಿಯಂತೆ ಈ ಆದೇಶವನ್ನು ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಪ್ರಶಾಂತ್‌ಕುಮಾರ್ ಎಸ್.ಬಿ.**

ಪಿ.ಆರ್. 1111

ಪೀಠಾಧಿಕಾರಿ–2

ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ

(ಇ–ಆಡಳಿತ)

## ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಸಚಿವಾಲಯ

## ತಿದ್ದುಪಡಿ

ಸಂಖ್ಯೆ: ಸಿಆಸುಇ 142 ಎಸ್‌ಇಎನ್ 2005, ಬೆಂಗಳೂರು, ದಿನಾಂಕ: 5–04–2012

ಶ್ರೀ ಬಿ.ಸಿ. ಮುಧೋಳ್, ನಿವೃತ್ತ ಮುಖ್ಯ ಇಂಜಿನಿಯರ್, ಇವರನ್ನು ಇವರ ವಿರುದ್ಧದ ಆರೋಪಗಳಿಂದ ಮುಕ್ತರನ್ನಾಗಿಸಿ ಹೊರಡಿಸಿರುವ ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 142 ಎಸ್‌ಇಎನ್ 2005ರಲ್ಲಿ ನಮೂದಿಸಿರುವ ಆದೇಶ ದಿನಾಂಕ: 08–03–2013ಅನ್ನು "08–03–2012" ಎಂದು ತಿದ್ದಿ ಓದಿಕೊಳ್ಳತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಎ.ಆರ್. ವಿಜಯಾನಂದ ಶರ್ಮ**

ಪಿ.ಆರ್. 1112

ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ

(ಸೇವೆಗಳು–3)

## ಆರ್ಥಿಕ ಸಚಿವಾಲಯ

**ವಿಷಯ:** ಕರ್ನಾಟಕ ರಾಜ್ಯ ಪಾನೀಯ ನಿಗಮ ನಿಯಮಿತದ ಮಾರ್ಜಿನ್ (ಒಚಿಡಿರುಟಿ) ನಿಗದಿಪಡಿಸುವ ಬಗ್ಗೆ.

**ಪ್ರಸ್ತಾವನೆ:**

2012–13ನೇ ಸಾಲಿನ ಆಯವ್ಯಯ ಭಾಷಣದ ಕಂಡಿಕೆ 273 ರಲ್ಲಿ ಕರ್ನಾಟಕ ರಾಜ್ಯ ಪಾನೀಯ ನಿಗಮ ನಿಯಮಿತದ ಮಾರ್ಜಿನ್ ಅನ್ನು ಶೇಕಡ 0.5ಕ್ಕೆ ಕಡಿಮೆಗೊಳಿಸುವುದಾಗಿ ಘೋಷಿಸಲಾಗಿರುತ್ತದೆ. ಈ ಹಿನ್ನೆಲೆಯಲ್ಲಿ ಈ ಕೆಳಕಂಡ ಆದೇಶ.

**ಸರ್ಕಾರದ ಆದೇಶ ಸಂಖ್ಯೆ: ಆಇ 03 ಪಿಇಎಸ್ 2012, ಬೆಂಗಳೂರು, ದಿನಾಂಕ 31–03–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಹಿನ್ನೆಲೆಯಲ್ಲಿ ಸರ್ಕಾರವು, ಡಿಸ್ಟ್ರಿಬ್ಯೂಟರ್ ಸನ್ನದುದಾರರಾದ ಕರ್ನಾಟಕ ರಾಜ್ಯ ಪಾನೀಯ ನಿಗಮ ನಿಯಮಿತವು ದಿನಾಂಕ: 01–04–2012 ರಿಂದ ಜಾರಿಗೆ ಬರುವಂತೆ ಮದ್ಯದ ಮೂಲ ಬೆಲೆಯ ಮೇಲೆ ಶೇಕಡ 0.5ನ್ನು ಮಾರ್ಜಿನ್ (ಒಚಿಡಿರುಟಿ) ಆಗಿ ವಿಧಿಸತಕ್ಕದ್ದೆಂದು ನಿಗದಿಪಡಿಸಿದೆ.

ಕರ್ನಾಟಕ ರಾಜ್ಯ ಪಾನೀಯ ನಿಗಮಕ್ಕೆ ವಿತರಕರ ಸನ್ನದು ಮಂಜೂರು ಮಾಡಿರುವುದಕ್ಕೆ ಕರ್ನಾಟಕ ರಾಜ್ಯ ಪಾನೀಯ ನಿಗಮವು ಸರ್ಕಾರಕ್ಕೆ ಪಾವತಿಸಬೇಕಾದ ಪ್ರಿವಿಲೇಜ್ ಫೀ ಬಗ್ಗೆ ಆದೇಶವನ್ನು ಪ್ರತ್ಯೇಕವಾಗಿ ಹೊರಡಿಸಲಾಗುವುದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಡಿ.ಎನ್. ವೆಂಕಟಚಲಪತಿ**

ಪಿ.ಆರ್. 1113

ಸರ್ಕಾರದ ಅಧೀನ ಕಾರ್ಯದರ್ಶಿ,

ಆರ್ಥಿಕ ಇಲಾಖೆ, (ಅಬಕಾರಿ)

## ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಸಚಿವಾಲಯ

**ವಿಷಯ:** ಸಿಆಸು ಇಲಾಖೆಯ ಆಡಳಿತ ಕೋಶ ಶಾಖೆಯಲ್ಲಿ ಒಂದು ಕಿರಿಯ ಸಹಾಯಕರ ಹುದ್ದೆಯನ್ನು ನೂತನವಾಗಿ ಸೃಜಿಸುವ ಬಗ್ಗೆ.

**ಓದಲಾಗಿದೆ:** ಅನಧಿಕೃತ ಟಿಪ್ಪಣಿ ಸಂಖ್ಯೆ:ಸಿಆಸುಇ 61 ಅಕೋ 2012; ದಿ: 24/01/2012 ಮತ್ತು ದಿ: 23/02/2012.

**ಪ್ರಸ್ತಾವನೆ:**

ಮೇಲೆ ಓದಲಾದ ಅನಧಿಕೃತ ಟಿಪ್ಪಣಿಯಲ್ಲಿ ಸಿಆಸು ಇಲಾಖೆಯ ಆಡಳಿತ ಕೋಶ ಶಾಖೆಯು ಸದರಿ ಶಾಖೆಯಲ್ಲಿ ಬಿ, ಸಿ ಹಾಗೂ ಡಿ ವೃಂದದ ಅಧಿಕಾರಿ: ನೌಕರರ ಇಲಾಖಾ ವಿಚಾರಣೆ: ಸಂಬಂಧಿತ ನ್ಯಾಯಾಲಯ ಪ್ರಕರಣ ಹಾಗೂ ಸಚಿವಾಲಯದ ಎಲ್ಲ ವೃಂದಗಳ ಜೇಷ್ಠತಾ ಪಟ್ಟಿ ತಯಾರಿಕೆಯಂಥ ಜವಾಬ್ದಾರಿಯುತ ಕಾರ್ಯ ನಿರ್ವಹಿಸುತ್ತಿದ್ದು, ಶಾಖೆಯಲ್ಲಿ ಕಿರಿಯ ಸಹಾಯಕರ ವೃಂದದ ಹುದ್ದೆ ಮಂಜೂರಾಗಿಲ್ಲದಿರುವುದರಿಂದ ಶಾಖೆಯಲ್ಲಿ ಸ್ವೀಕೃತ ಹಾಗೂ ರವಾನೆ ಕಾರ್ಯ ನಿರ್ವಹಣೆಗೆ ತೀವ್ರ ಅಡಚಣೆಯಾಗಿದೆ ಎಂದು ವಿವರಿಸಲಾಗಿದೆ. ಈ ಸಂಬಂಧ ಒಂದು ಕಿರಿಯ ಸಹಾಯಕರ ಹುದ್ದೆಯನ್ನು ಸೃಜಿಸಲು ಕೋರಲಾಗಿದೆ.

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ, ಈ ಕೆಳಕಂಡಂತೆ ಆದೇಶಿಸಲಾಗಿದೆ

**ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 21 ಆಕಿಸೇ 2012, ಬೆಂಗಳೂರು, ದಿನಾಂಕ 10–04–2012**

ಕರ್ನಾಟಕ ಸರ್ಕಾರ ಸಚಿವಾಲಯದ ಸಿಆಸು ಇಲಾಖೆಯ ಆಡಳಿತ ಕೋಶ ಶಾಖೆಯಲಿ ಒಂದು ಕಿರಿಯ ಸಹಾಯಕರ ಹುದ್ದೆಯನ್ನು ಶಾಶ್ವತವಾಗಿ ಸೃಜಿಸಲು ಹಾಗೂ ವೃಂದದಲ್ಲಿ ಚಾಲ್ತಿ ಕಾರ್ಯನಿರ್ವಹಿಸುತ್ತಿರುವ ಕಿರಿಯ ಸಹಾಯಕರಿಂದಲೇ ಭರ್ತಿ ಮಾಡಲು ಮಂಜೂರಾತಿಯನ್ನು ನೀಡಲಾಗಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯು ಟಿಪ್ಪಣಿ ಸಂಖ್ಯೆ: ಆಇ 229 ವೆಚ್ಚ–12/2012; ದಿ: 28/03/2012ರಲ್ಲಿ ನೀಡಿರುವ ಸಹಮತಿಯನುಸಾರ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಜೋಸ್ ಗ್ಸೇವಿಯರ್**

ಪಿ.ಆರ್. 1114

ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಆಸು ಇಲಾಖೆ (ಆಡಳಿತ–2)

## ಕಂದಾಯ ಸಚಿವಾಲಯ

**ವಿಷಯ:** ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ವಾರ್ಡ್ ನಂ. 23 ಬೆಂಗಳೂರು ಉತ್ತರ ತಾಲ್ಲೂಕು, ಕಸಬಾ ಹೋಬಳಿ, ನಾಗಾವಾರ ಗ್ರಾಮದ ಸರ್ವೆ ನಂ. –50/ಎ ಮತ್ತು 158 ರಲ್ಲಿ ಅನುಕ್ರಮವಾಗಿ 3266.98 ಚ. ಅಡಿ ಮತ್ತು 2178 ಚ. ಅಡಿ ಜಮೀನಿನ ಜಾಗವನ್ನು ವಿಶೇಷ ವಿತ್ತಿ ವಲಯಕ್ಕೆ (ಖಇಚ) ಸಂಪರ್ಕ ರಸ್ತೆ ಕಲ್ಪಿಸುವ ಸಲುವಾಗಿ ಭೂಸ್ವಾಧೀನಪಡಿಸಿಕೊಳ್ಳಲು ಭೂಸ್ವಾಧೀನ ಕಾಯ್ದೆಯ ಕಲಂ 6(1)ರ ಪ್ರಕಾರ ಅಂತಿಮ ಅಧಿಸೂಚನೆ.

**ಓದಲಾಗಿದೆ:**

1) 1894ರ ಭೂಸ್ವಾಧೀನ ಅಧಿನಿಯಮ (ತಿದ್ದುಪಡಿಯಾದ 1991ರ ಕರ್ನಾಟಕ ಅಧಿನಿಯಮ 33) ರ ಪ್ರಕಾರ ಕಲಂ 4(1)ಕ್ಕೆ ಅನುಸಾರವಾಗಿ ಹೊರಡಿಸಲಾಗಿರುವ 26–05–2011 ರ ದಿನಾಂಕದ ಕರ್ನಾಟಕ ರಾಜ್ಯ ಪತ್ರ 3ನೇ ಭಾಗ ಪುಟ 1663 ರಲ್ಲಿ ಪ್ರಕಟವಾಗಿರುವ ಕ್ರಮಾಂಕ: ಎಲ್ಎಕ್ಯೂ/ಸಿಆರ್/40/2009–10 ದಿನಾಂಕ 13–05–2011 ರ ಅಧಿಸೂಚನೆ.

2) ಜಂಟಿ ಆಯುಕ್ತರು (ಭೂಸ್ವಾಧೀನ) ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ಇವರ ಪತ್ರ ಸಂಖ್ಯೆ: ಎಲ್ಎಕ್ಯೂ/ಸಿಆರ್/40/2009–10, ದಿನಾಂಕ: 07–03–2012.

**ಸರ್ಕಾರಿ ಆದೇಶ ಸಂಖ್ಯೆ: ಕಂಇ 204 ಭೂಸ್ವಾಬೆ 2011 ಬೆಂಗಳೂರು, ದಿನಾಂಕ 09–04–2012**

1894ರ ಭೂಸ್ವಾಧೀನ ಅಧಿನಿಯಮದ ಪ್ರಕರಣ 6(1–ಎ)ರ ಮೇರೆಗೆ ಮುಂದುವರೆಯಲು ನೀಡಲಾದ ನಿರ್ದೇಶನವನ್ನು ಅನುಸರಿಸಿ ಬಂದಿರುವ ವರದಿಯನ್ನು ಪರಿಶೀಲಿಸಿ ಕರ್ನಾಟಕ ಸರ್ಕಾರ ಸಾರ್ವಜನಿಕ ಉದ್ದೇಶಕ್ಕೆ ಅಂದರೆ ಸಂಪರ್ಕ ರಸ್ತೆ ಕಲ್ಪಿಸುವ ಸಲುವಾಗಿ ಒಟ್ಟು 5445 ಚದರ ಅಡಿಗಳು ಜಮೀನು ಅಗತ್ಯವಾಗಿದೆ ಎಂಬುದನ್ನು ಮನಗಂಡಿದೆ. ಸದರಿ ಅಧಿನಿಯಮದ 6ನೇ ಪ್ರಕರಣದ ಮೇರೆಗೆ ಜಂಟಿ ಆಯುಕ್ತರು (ಭೂಸ್ವಾಧೀನ)

ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ, ಇವರನ್ನು ಜಿಲ್ಲಾಧಿಕಾರಿಗಳ ಕಾರ್ಯವನ್ನು ನಿರ್ವಹಿಸಲು ನೇಮಿಸಲಾಗಿದೆ. ಮತ್ತು ಸ್ವತ್ತುಗಳನ್ನು ಸ್ವಾಧೀನಪಡಿಸಲು ಆದೇಶಿಸುವ ಅಧಿಕಾರವನ್ನು ನೀಡಲಾಗಿದೆ. ಕರಡು ಐತೀರ್ಪು ರಚಿಸುವ ಮುನ್ನಾ ಭೂಸ್ವಾಧೀನ ವೆಚ್ಚದ ಪೂರ್ಣ ಮೊತ್ತವನ್ನು ಸಂಬಂಧಿಸಿದ ಇಲಾಖೆಯಿಂದ ಭರಣ ಮಾಡಿಕೊಳ್ಳತಕ್ಕದ್ದು. ಈ ಪ್ರಕರಣದಲ್ಲಿ ಕಲಂ 6(1)ರ ರೀತ್ಯಾ ಅಧಿಸೂಚನೆ ಹೊರಡಿಸಿದೆ.

1894ರ ಭೂಸ್ವಾಧೀನ ಕಾಯ್ದೆಯ (ತಿದ್ದುಪಡಿಯಾದ 1991ರ ಕರ್ನಾಟಕ ಕಾಯ್ದೆ 33) 6ನೇ ಕಲಂಗೆ ಅನುಗುಣವಾಗಿ ಅನುಮೋದಿಸಲಾದ ಅಧಿಸೂಚನೆ ಪ್ರತಿಯನ್ನು ಅನುಬಂಧಿಸಿ ಪ್ರಕಟಣೆಗಾಗಿ ಉಪ ನಿರ್ದೇಶಕರು, ಸರ್ಕಾರಿ ಮುದ್ರಣಾಲಯ, ಹೊರವಲಯ, ಮೈಸೂರು ರಸ್ತೆ, ಬೆಂಗಳೂರು, ಇವರಿಗೆ ಕಳುಹಿಸಿದೆ.

ಈ ಉದ್ದೇಶಕ್ಕಾಗಿ ಕೊಡಲಾಗಿರುವ ಹಣದಿಂದ ಭೂಸ್ವಾಧೀನ ವೆಚ್ಚವನ್ನು ಭರಿಸತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಎಂ. ವೆಂಕಟೇಶಮೂರ್ತಿ**

ಸರ್ಕಾರದ ಅಧೀನ ಕಾರ್ಯದರ್ಶಿ,

ಕಂದಾಯ ಇಲಾಖೆ (ಭೂಸ್ವಾ–2)

**ಭೂಸ್ವಾಧೀನ ಅಧಿನಿಯಮ 6(1)ನೇ ಪ್ರಕರಣದ ಮೇರೆಗೆ ಘೋಷಣೆ**

**ಅಧಿಸೂಚನೆ ಸಂಖ್ಯೆ: ಕಂಇ 204 ಭೂಸ್ವಬೆ 2011 ದಿನಾಂಕ: 9–4–2012**

ಇದರ ಅನುಸೂಚಿಯಲ್ಲಿ ನಿರ್ದಿಷ್ಟಪಡಿಸಿರುವ ಜಮೀನುಗಳನ್ನು ಸಾರ್ವಜನಿಕ ಉದ್ದೇಶಕ್ಕಾಗಿ ಅಂದರೆ ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ಬರುವ ವಾರ್ಡ್ ಸಂಖ್ಯೆ: 23, ಬೆಂಗಳೂರು ಉತ್ತರ ತಾಲ್ಲೂಕು, ಕಸಬಾ ಹೋಬಳಿ, ನಾಗವಾರ ಗ್ರಾಮದ ಸರ್ವೆ ನಂ–50/1ಎ ಮತ್ತು ಸರ್ವೆ ನಂ–158 ರಲ್ಲಿ ಅನುಕ್ರಮವಾಗಿ 3266.98 ಚ.ಅ. ಮತ್ತು 2178 ಚ.ಡಿ. ಜಮೀನಿನ ಜಾಗವನ್ನು ವಿಶೇಷ ವಿತ್ತ ವಲಯಕ್ಕೆ (SEZ) ಸಂಪರ್ಕ ಕಲ್ಪಿಸಲು ಭೂಸ್ವಾಧೀನ ಕಾಯ್ದೆ 1894ರ ಕಲಂ 4(1)ರ ಮೇರೆಗೆ ಕ್ರಮಾಂಕ: ಎಲ್‌ಎಕ್ಯೂ/ಸಿಆರ್/40/2009–10, ದಿನಾಂಕ: 13–05–2011 ರಂದು ಹೊರಡಿಸಲಾಗಿದೆ ಅಧಿಸೂಚನೆಯು ಕರ್ನಾಟಕ ರಾಜ್ಯಪತ್ರದಲ್ಲಿ ದಿನಾಂಕ: 26–05–2011 ರಂದು ಅಧಿಸೂಚಿಸಲಾಗಿದ್ದುದರಿಂದ,

ಮತ್ತು ಕರ್ನಾಟಕ ಕಾಯ್ದೆ 33–1991 ರನ್ವಯ ತಿದ್ದುಪಡಿಯಾದ ಭೂ ಅರ್ಜನೆ ಅಧಿನಿಯಮ 1894 (ಕೇಂದ್ರ ಅಧಿನಿಯಮ ಸಂಖ್ಯೆ: 1894) ರ 5–ಎ ಪ್ರಕರಣದ, (2) ನೇ ಉಪ ಪ್ರಕರಣದ ಮತ್ತು 6(1ಎ) ಪ್ರಕರಣದ ಮೇರೆಗೆ ಜಂಟಿ ಆಯುಕ್ತರು (ಭೂಸ್ವಾಧೀನ), ಬೃಹತ್ ಬೆಂಗಳೂರು ಮಹಾನಗರ ಪಾಲಿಕೆಯವರು ನೀಡಿರುವ ವರದಿಯನ್ನು ಪರಿಶೀಲಿಸಿದ ನಂತರ, ಮೇಲೆ ನಿರ್ದಿಷ್ಟಪಡಿಸಿದ ಉದ್ದೇಶಕ್ಕಾಗಿ ಸದರಿ ಭೂಮಿಗಳನ್ನು ಅರ್ಜನೆ ಮಾಡಿಕೊಳ್ಳುವ ಅಗತ್ಯವಿದೆ ಎಂದು ಕರ್ನಾಟಕ ಸರ್ಕಾರಕ್ಕೆ ಮನದಟ್ಟಾಗಿರುವುದರಿಂದ,

ಮೇಲೆ ತಿಳಿಸಿದ ಉದ್ದೇಶಕ್ಕಾಗಿ ಭೂಮಿಗಳು ಅಗತ್ಯವಾಗಿವೆ ಎಂದು ಸದರಿ ಅಧಿನಿಯಮದ 6(1)ನೇ ಪ್ರಕರಣದ ಮೇರೆಗೆ ಈ ಮೂಲಕ ಘೋಷಿಸಲಾಗಿದೆ.

ವಿಶೇಷ ಭೂಸ್ವಾಧೀನಾಧಿಕಾರಿಗಳು ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ, ಬೆಂಗಳೂರು ಇವರನ್ನು ಸದರಿ ಭೂಮಿಗಳಿಗೆ ಸಂಬಂಧಿಸಿದಂತೆ ಇನ್ನು ಮುಂದೆ ಕೈಗೊಳ್ಳುವ ಎಲ್ಲಾ ವ್ಯವಹಾರಗಳ ಕುರಿತಂತೆ ಜಂಟಿ ಆಯುಕ್ತರು (ಭೂಸ್ವಾಧೀನ) ರವರ ಪ್ರಕಾರ್ಯಗಳನ್ನು ನಿರ್ವಹಿಸುವ ಸಲುವಾಗಿ ಸದರಿ ಭೂ ಅರ್ಜನೆ ಅಧಿನಿಯಮದ 3ನೇ ಪ್ರಕರಣದ (ಸಿ) ಖಂಡದ ಮೇರೆಗೆ ನೇಮಕ ಮಾಡಲಾಗಿದೆ ಹಾಗೂ ಸದರಿ ಭೂಮಿಯ ಅರ್ಜನೆಗೆ ಸಂಬಂಧಿಸಿದ ಆದೇಶವನ್ನು ಪಡೆದುಕೊಳ್ಳುವ ಸದರಿ ಅಧಿನಿಯಮದ 7ನೇ ಪ್ರಕರಣದ ಮೇರೆಗೆ ನಿರ್ದೇಶನ ನೀಡಲಾಗಿದೆ. ಸದರಿ ಭೂಮಿಗಳ ನಕಾಶೆಯನ್ನು ಪರಿವೀಕ್ಷಣೆಗಾಗಿ ವಿಶೇಷ ಭೂಸ್ವಾಧೀನಾಧಿಕಾರಿಗಳು, ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ, ಬೆಂಗಳೂರು. ಇವರ ಕಛೇರಿಯಲ್ಲಿ ಇಡಲಾಗಿದೆ.

**ಅನುಸೂಚಿ**

ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ಬರುವ ವಾರ್ಡ್ ಸಂಖ್ಯೆ: 23 ಬೆಂಗಳೂರು ಉತ್ತರ ತಾಲ್ಲೂಕು, ಕಸಬಾ ಹೋಬಳಿ, ನಾಗವಾರ ಗ್ರಾಮದ ಸರ್ವೆ ನಂ. 50/1ಎ ಮತ್ತು 158 ರಲ್ಲಿ ಅನುಕ್ರಮವಾಗಿ 3266.98 ಚ.ಅಡಿ ಮತ್ತು 2178 ಚ.ಅಡಿ ಜಮೀನಿನ ಜಾಗವನ್ನು ವಿಶೇಷ ವಿತ್ತವಲಯಕ್ಕೆ (SEZ) ಸಂಪರ್ಕ ರಸ್ತೆ ನಿರ್ಮಾಣಕ್ಕಾಗಿ ಭೂಸ್ವಾಧೀನಪಡಿಸಿಕೊಳ್ಳುತ್ತಿದ್ದು, ಸದರಿ ಜಾಗದ ವಿವರಗಳು ಈ ಕೆಳಕಂಡಂತೆ ಇದೆ:

| ಕ್ರ.ಸಂ. | ಆರ್.ಟಿ.ಸಿ. ಯಂತೆ ಖಾತೆದಾರರ ಹೆಸರು | ಅನುಭವದಾರರ/ ಅಕ್ಷೇಪಣೆದಾರರ ಹೆಸರು | ಗ್ರಾಮದ ಹೆಸರು/ ಸರ್ವೆ ನಂ. | ತರಹೆ | ಚಕ್ಕುಬಂದಿ | | | | ಭೂಸ್ವಾಧೀನ ಪಡಿಸಿಕೊಳ್ಳುತ್ತಿರುವ ವಿಸ್ತೀರ್ಣ ಚ.ಅ.ಗಳಲ್ಲಿ |
|---|---|---|---|---|---|---|---|---|---|
| | | | | | ಪೂರ್ವ | ಪಶ್ಚಿಮ | ಉತ್ತರ | ದಕ್ಷಿಣ | |
| 1 | 2 | 3 | 4 | 5 | 6 | 7 | 8 | 9 | 10 |
| 1. | 1. ಚಿಕ್ಕಕರುಗಪ್ಪ<br>2. ರಾಮಚಂದ್ರಪ್ಪ<br>3. ರಾಮಣ್ಣ<br>4. ಸತ್ಯನಾರಾಯಣ<br>5. ಎಂ. ವೆಂಕಟರಾಮಯ್ಯ<br>6. ತ್ರಿಲೋಕ್ಯನಾಥ | 1) ಬರ್ತ್‌ಲೋಮ್ ಉ॥ ಬಿ.ಸಿ. ರೆಡ್ಡಿ ಬಿನ್ ಲೇ॥ ಡಿ. ಚೌರಪ್ಪ<br>2) ಪಿ.ಆರ್. ಮೇರಿ ಜಯಶ್ರೀ ಕೋಂ ಲೇ॥ ಅಂಥೋಣಿ ಸ್ವಾಮಿ ಉರುಫ್ ಸಿ. ಪ್ಯಾಟ್ರಿಕ್ | ನಾಗವಾರ 50/1ಎ | ಖಾಲಿ ಜಾಗ ಮತ್ತು ಶೀಟ್ ವರ್ಕ್‌ಷಾಪ್ ಕಟ್ಟಡ ಆರ್.ಸಿ.ಸಿ. ಹೋಟೆಲ್ | ಸರ್ವೆ ನಂ. 73/1 | 50/1ಎ ರ ಉಳಿಕೆ | 158 | ಹೊರ ವರ್ತುಲ ರಸ್ತೆ | 3267 |

| | | | | | | | | | |
|---|---|---|---|---|---|---|---|---|---|
| | 7. ಬರ್ತ್‌ಲೋಮ್ ಉ॥ ಬಿ.ಸಿ. ರೆಡ್ಡಿ ಬಿನ್ ಚೌರಪ್ಪ<br>8. ಪಿ.ಆರ್. ಮೇರಿ ಜಯಶ್ರೀ, ಕೋಂ ಲೇ॥ ಅಂಥೋಣಿ ಸ್ವಾಮಿ ಉರುಫ್ ಸಿ. ಪ್ಯಾಟ್ರಿಕ್<br>9. ಶ್ರೀಮತಿ ಉಮಾ. ಎನ್. ಕೋಂ. ಡಿ. ಗಣೇಶ್ | 3) ಸತ್ಯನಾರಾಯಣ<br>4) ಎಂ. ವೆಂಕಟರಾಮಯ್ಯ<br>5) ಶ್ರೀಮತಿ ಉಮಾ ಎನ್. ಕೋಂ ಡಿ. ಗಣೇಶ್<br>6) ಸಿ. ಕಾಂತರಾಜ್ ಬಿನ್ ಲೇ॥ ಡಿ. ಚೌರಪ್ಪ | | ಕಟ್ಟಡ ಶೀಟ್ ಮನೆ | | | | | |
| 2. | 1) ಪಿ. ಮುನಿರಾಮಯ್ಯ ಬಿನ್ ಪಿಲ್ಲಣ್ಣ<br>2) ಪಿ. ಮುನಿನಂಜಪ್ಪ ಬಿನ್ ಪಿಲ್ಲಣ್ಣ<br>3) ಪಿ. ಚನ್ನಪ್ಪ ಬಿನ್ ಪಿಲ್ಲಣ್ಣ<br>4) ಮುದ್ದಮ್ಮ ಕೋಂ ಪಿಲ್ಲಣ್ಣ<br>5) ಪಿ. ನಾರಾಯಣ ಬಿನ್ ಪಿಲ್ಲಣ್ಣ<br>6) ಪಿ. ಶಿವಶಂಕರ್ ಪಿಲ್ಲಣ್ಣ<br>7) ಗೋಪಾಲ ಬಿನ್ ಪಿಲ್ಲಣ್ಣ<br>8) ಬಿ. ಶ್ರೀನಿವಾಸ ಬಿನ್ ಪಿಲ್ಲಣ್ಣ | 1) ಪಿ. ಮುನಿರಾಮಯ್ಯ ಬಿನ್ ಪಿಲ್ಲಣ್ಣ<br>2) ಪಿ. ಮುನಿನಂಜಪ್ಪ ಬಿನ್ ಪಿಲ್ಲಣ್ಣ<br>3) ಪಿ. ಚನ್ನಪ್ಪ ಬಿನ್ ಪಿಲ್ಲಣ್ಣ<br>4) ಮುದ್ದಮ್ಮ ಕೋಂ ಪಿಲ್ಲಣ್ಣ<br>5) ಪಿ. ನಾರಾಯಣ ಬಿನ್ ಪಿಲ್ಲಣ್ಣ<br>6) ಗೋಪಾಲ ಬಿನ್ ಪಿಲ್ಲಣ್ಣ<br>7) ಪಿ. ಶಿವಶಂಕರ್ ಪಿಲ್ಲಣ್ಣ<br>8) ಬಿ. ಶ್ರೀನಿವಾಸ ಬಿನ್ ಪಿಲ್ಲಣ್ಣ | ನಾಗವಾರ 158 | ಖುಷ್ಕಿ/ ಖಾಲಿ ಜಾಗ | ಸರ್ವೆ ನಂ. 73/1 | ಕೆರೆ | ಸರ್ವೆ ನಂ. 61/2 | 50/1ಎ | 2178 |
| | | | | | | | | **ಒಟ್ಟು ವಿಸ್ತೀರ್ಣ (ಚ.ಅ.ಗಳಲ್ಲಿ)** | **5445** |

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ
**ಎಂ. ವೆಂಕಟೇಶಮೂರ್ತಿ**
ಸರ್ಕಾರದ ಅಧೀನ ಕಾರ್ಯದರ್ಶಿ,
ಕಂದಾಯ ಇಲಾಖೆ (ಭೂಸ್ವಾ–2 ಮತ್ತು ಪುನರ್ವಸತಿ)

ಪಿ.ಆರ್. 1115

## ಜಲಸಂಪನ್ಮೂಲ ಸಚಿವಾಲಯ

**ವಿಷಯ:** ಹಾವೇರಿ ಜಿಲ್ಲೆ, ಹಾವೇರಿ ತಾಲ್ಲೂಕು, ದಿಡಗೂರು ಸಣ್ಣ ನೀರಾವರಿ ಕೆರೆ ನಿರ್ಮಾಣ ಕಾಮಗಾರಿಗಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ನ್ಯಾಯಾಲಯದ ಆದೇಶಾನುಸಾರ ಹೆಚ್ಚುವರಿ ಪರಿಹಾರ ಧನ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ (ಉತ್ತರ) ವಲಯ, ಬಿಜಾಪುರ ಇವರ ದಿನಾಂಕ 06.08.2011 ರ ಪತ್ರ ಸಂಖ್ಯೆ: ಮುಇಂ/ಸನೀ/(ಉ)ವ/ಬೀಜಾ/ಭೂಸ್ವಾಪ್ರ/2011–12/4218.

**ಪ್ರಸ್ತಾವನೆ:**

ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ (ಉತ್ತರ) ವಲಯ, ಬಿಜಾಪುರ ಇವರು ಮೇಲೆ ಓದಲಾದ ದಿನಾಂಕ: 06–08–2011ರ ಪತ್ರದಲ್ಲಿ ಹಾವೇರಿ ಜಿಲ್ಲೆ ಹಾವೇರಿ ತಾಲ್ಲೂಕು ದಿಡಗೂರು ಸಣ್ಣ ನೀರಾವರಿ ಕೆರೆ ಕಾಲುವೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ದಿಡಗೂರು ಗ್ರಾಮದ ಜಮೀನುಗಳಿಗೆ ನ್ಯಾಯಾಲಯವು ನೀಡಿರುವ ತೀರ್ಪಿನನುಸಾರ ಹೆಚ್ಚುವರಿ ಪರಿಹಾರ ಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿರುತ್ತಾರೆ. ಹೆಚ್ಚುವರಿ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನ ಪ್ರಕ್ರಿಯೇ ವಿವರಗಳು ಈ ಕೆಳಕಂಡಂತಿವೆ.

- ಕರ್ನಾಟಕ ಭೂಸ್ವಾಧೀನ ಕಾಯ್ದೆ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 30–04–1987.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 11(ಎ)ರಡಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ರಚಿಸಿದ ದಿನಾಂಕ: 03–10–1988.

ಭೂಸ್ವಾಧೀನಕ್ಕೊಳಪಟ್ಟ ದಿಡಗೂರು ಗ್ರಾಮದ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳು ರಚಿಸಿದ ಪರಿಹಾರಧನದ ಐತೀರ್ಪಿನಂತೆ ಹಣ ಪಡೆದು ಇನ್ನೂ ಹೆಚ್ಚಿನ ಪರಹಾರ ನೀಡುವಂತೆ ಭೂಸ್ವಾಧೀನ ಕಾಯ್ದೆ 1894 ಕಲಂ 18(1)ರಡಿ ಹಾವೇರಿ (ಹಿರಿಯ ಶ್ರೇಣಿ) ಸಿವಿಲ್ ನ್ಯಾಯಾಲಯದಲ್ಲಿ ಭೂಸ್ವಾಧೀನ ಪ್ರಕರಣ ಸಂಖ್ಯೆ: 26/90 ನ್ನು ದಾಖಲಿಸಿದ್ದು. ಈ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಹಾಗೂ ಸದರಿ ಜಮೀನುಗಳನ್ನು ಕಬ್ಜೆ ಪಡೆದ ದಿನಾಂಕ 04–10–1960 ರಿಂದ ಬಡ್ಡಿ ಪಾವತಿಸುವಂತೆ ಆದೇಶಿಸಿ ದಿನಾಂಕ 13–11–1990 ರಂದು ತೀರ್ಪು ನೀಡಿದೆ. ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಭೂಸ್ವಾಧೀನಾಧಿಕಾರಿಗಳು ಉಚ್ಚ ನ್ಯಾಯಾಲಯದಲ್ಲಿ ಮೇಲ್ಮನವಿ ಸಲ್ಲಿಸಿದ್ದು, ಉಚ್ಚ ನ್ಯಾಯಾಲಯವು ಸಿವಿಲ್ ನ್ಯಾಯಾಲಯ ನೀಡಿದ ತೀರ್ಪನ್ನು ಭಾಗಶಃ ಮಾರ್ಪಡಿಸಿ, ಪುರಸ್ಕರಿಸಿರುತ್ತದೆ. ಈ ತೀರ್ಪಿನ ವಿರುದ್ಧ ಪುನಃ ಉಚ್ಚ ನ್ಯಾಯಾಲಯದಲ್ಲಿ ರಿಟ್ ಅಪೀಲ್ ಸಲ್ಲಿಸಿದ್ದು, ಅದೂ ಸಹ ವಜಾಗೊಂಡಿರುತ್ತದೆ.

ಸಿವಿಲ್ ನ್ಯಾಯಾಲಯವು ಹೆಚ್ಚುವರಿ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣದ ವಿವರ ಈ ಕೆಳಕಂಡಂತಿದೆ.

(ರೂ.ಗಳಲ್ಲಿ)

| ಕ್ರಮ ಸಂಖ್ಯೆ | ಎಲ್.ಎ.ಸಿ. ಸಂಖ್ಯೆ | ದಿಡಗೂರು ಗ್ರಾಮದ ಸರ್ವೆ ನಂಬರ್ | ವಿಸ್ತೀರ್ಣ ಎ–ಗುಂ | ಪರಿಹಾರ ಧನದ ಮೊತ್ತ |
|---|---|---|---|---|
| 1 | 26/90 | 1645/91 | 2–12 | 14,39,624–00 |
| • ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ | | | | |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ, ಸರ್ಕಾರವು ಈ ಕೆಳಕಂಡಂತೆ ಅದೇಶ ಹೊರಡಿಸಿದೆ

**ಸರ್ಕಾರದ ಆದೇಶ ಸಂಖ್ಯೆ: ಸನೀಇ 109 ಭೂಸ್ವಾಪ್ರ 2011, ಬೆಂಗಳೂರು, ದಿನಾಂಕ 30–03–2012**

ಹಾವೇರಿ ಜಿಲ್ಲೆ, ಹಾವೇರಿ ತಾಲ್ಲೂಕು, ದಿಡಗೂರು ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ದಿಡಗೂರು ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ನ ಜಮೀನಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿದ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಹಾಕಿದ ಪರಿಹಾರ ಮೊತ್ತ ರೂ. 14,39,624–00 (ಹದಿನಾಲ್ಕು ಲಕ್ಷದ ಮೂವತ್ತೊಂಭತ್ತು ಸಾವಿರದ ಆರು ನೂರ ಇಪ್ಪತ್ನಾಲ್ಕು ರೂಪಾಯಿಗಳು ಮಾತ್ರ) ಗಳನ್ನು ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–0–800–1–00 ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗ್ಗೆ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 01 ಟಿಎಫ್‌ಪಿ 2010, ದಿನಾಂಕ 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ. ಸಿ. ಸಿದ್ದಪ್ಪ**

ಪಿ.ಆರ್. 1116

ಸರ್ಕಾರದ ಅಧೀನ ಕಾರ್ಯದರ್ಶಿ,

ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ಹಿರೇಕೊಪ್ಪ ಗ್ರಾಮದ ಹದ್ದಿನಲ್ಲಿ ಬಸಿ ನೀರಿನ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ : ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011–12/6159, ದಿನಾಂಕ : 05–12–2011.

**ಪ್ರಸ್ತಾವನೆ :**

ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ಹಿರೇಕೊಪ್ಪ ಗ್ರಾಮದ ಹದ್ದಿನಲ್ಲಿ ಬಸಿ ನೀರಿನ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಹಿರೇಕೊಪ್ಪ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣದಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ದಿನಾಂಕ : 05–12–2011ರ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ.

ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರ ಅಧಿಸೂಚನೆಯನ್ನು ದಿನಾಂಕ : 06–09–07ರಂದು ಹೊರಡಿಸಿದೆ. ಭೂಸ್ವಾಧೀನಾಧಿಕಾರಿಗಳು ದಿನಾಂಕ : 30–05–09ರಂದು ರಚಿಸಿದ ಐತೀರ್ಪಿನಲ್ಲಿ ಪ್ರತಿ ಎಕರೆಗೆ ರೂ. 21,000/–ಗಳ ಮಾರುಕಟ್ಟೆ ಬೆಲೆ ನಿಗದಿಪಡಿಸಿರುತ್ತಾರೆ. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ರಾಮದುರ್ಗ ಸಿವಿಲ್ (ಹಿರಿಯ ವಿಭಾಗ) ನ್ಯಾಯಾಲಯದಲ್ಲಿ ಎಲ್.ಎ.ಸಿ.

ಪ್ರಕರಣಗಳನ್ನು ದಾಖಲಿಸಿದ್ದು, ನ್ಯಾಯಾಲಯವು ಪ್ರತಿ ಎಕರೆಗೆ ರೂ. 2,36,000/–ಗಳನ್ನು ನಿಗದಿಪಡಿಸಿದೆ. ಸಿವಿಲ್ ನ್ಯಾಯಾಲಯದ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯು ಪತ್ರ ಸಂಖ್ಯೆ : ಆರ್‌ಡಿ 242 ಎಲ್‌ಸಿಬಿ 20112, 07–03–12ರಲ್ಲಿ ಅಭಿಪ್ರಾಯ ನೀಡಿದೆ. ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ :

| ಕ್ರ. ಸಂ. | ಎಲ್‌ಎಸಿ | ಹಿರೇಕೊಪ್ಪ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|
| 1 | 30/10 | 43 | 10–32 | 46,15,650–00 |
| **ಒಟ್ಟು** | | | | **46,15,650–00** |

ಪ್ರಸ್ತಾವನೆಯಲ್ಲಿನ ಅಂಶಗಳನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ : ಸನೀಇ 178 ಭೂಸ್ವಾಪ್ರ 2011, ಬೆಂಗಳೂರು, ದಿನಾಂಕ : 30–03–2012**

ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ಹಿರೇಕೊಪ್ಪ ಗ್ರಾಮದ ಹದ್ದಿನಲ್ಲಿ ಬಸಿ ನೀರಿನ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಹಿರೇಕೊಪ್ಪ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ರೂ. 46,15,650–00 ಗಳನ್ನು (ನಲವತ್ತಾರು ಲಕ್ಷದ ಹದಿನೈದು ಸಾವಿರದ ಆರುನೂರ ಐವತ್ತು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

4. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
5. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
6. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 46,15,650/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕ ಪ್ರತ್ಯಾಯೋಜನೆಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಪಿ.ಆರ್. 1117 ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೆಳಗಾಂ ಜಿಲ್ಲೆ, ಸವದತ್ತಿ ತಾಲ್ಲೂಕು ಕೊಡ್ಲಿವಾಡ ಸತ್ತಿಗೇರಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ದಿನಾಂಕ : 31–10–2011ರ ಪತ್ರ ಸಂಖ್ಯೆ : ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011–12/5560, ದಿನಾಂಕ : 31–10–2011.

**ಪ್ರಸ್ತಾವನೆ :**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಬೆಳಗಾಂ ಜಿಲ್ಲೆ ಸವದತ್ತಿ ತಾಲ್ಲೂಕು ಕೊಡ್ಲಿವಾಡ ಸತ್ತಿಗೇರಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಸತ್ತಿಗೇರಿ ಹಾಗೂ ಕೊಡ್ಲಿವಾಡ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣದಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ :

– ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ : 18–11–2004.
– ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ : 25–05–2007.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಸವದತ್ತಿ ಸಿವಿಲ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಭೂಸ್ವಾಧೀನ ಪ್ರಕರಣಗಳನ್ನು ದಾಖಲಿಸಿದ್ದು, ಈ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದೆ. ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶವು ಪತ್ರ ಸಂಖ್ಯೆ : ಆರ್‌ಡಿ 651 ಎಲ್‌ಸಿಬಿ 2011, ದಿನಾಂಕ : 07–12–2011ರಲ್ಲಿ ಅಭಿಪ್ರಾಯ ನೀಡಿದೆ. ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ ;

| ಕ್ರ. ಸಂ. | ಎಲ್‌ಎಸಿ ಸಂಖ್ಯೆ | ಕೊಡ್ಲಿವಾಡ ಮತ್ತು ಸತ್ತಿಗೇರಿ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 46/09 | 752/1ಎ | 2–20 | 977706 |
| 2 | 47/09 | 752/1ಬಿ | 0–20 | 195941 |
| 3 | 51/09 | 758/1 | 0–35 | 342522 |
| | **ಒಟ್ಟು** | | | **15,16,169–00** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ : ಸನೀಇ 161 ಭೂಸ್ವಾಪ್ರ 2011, ಬೆಂಗಳೂರು, ದಿನಾಂಕ : 30–03–2012**

ಬೆಳಗಾಂ ಜಿಲ್ಲೆ ಸವದತ್ತಿ ತಾಲ್ಲೂಕು ಸತ್ತಿಗೇರಿ ಮತ್ತು ಕೊಡ್ಲಿವಾಡ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಸದರಿ ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಹಾಕಿದ ಪರಿಹಾರ ಧನ ಮೊತ್ತ ರೂ. 15,16,169–00ಗಳನ್ನು (ಹದಿನೈದು ಲಕ್ಷದ ಅದಿನಾರು ಸಾವಿರದ ಒಂದು ನೂರ ಅರವತ್ತೊಂಭತ್ತು ರೂ.ಗಳು ಮಾತ್ರ) ಪಾವತಿಸಲು ಸರ್ಕಾರ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

6. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
7. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
8. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ಭರಿಸತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಅಧಿಕಾರ ಪ್ರತ್ಯಾಯೋಜನೆಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಪಿ.ಆರ್. 1118 ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ಬಟಕುರ್ಕಿ ಹಾಗೂ ಚನ್ನಾಪೂರ ಗ್ರಾಮದ ಹದ್ದಿನಲ್ಲಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ದಿನಾಂಕ : 05–12–2011ರ ಪತ್ರ ಸಂಖ್ಯೆ : ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011–12/6149, ದಿನಾಂಕ : 05–12–11.

**ಪ್ರಸ್ತಾವನೆ :**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕಿನ ಬಟಕುರ್ಕಿ ಹಾಗೂ ಚನ್ನಾಪೂರ ಗ್ರಾಮಗಳ ಹದ್ದಿಯಲ್ಲಿ ರಾಜನಾಳ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ :

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ : 17–04–2003.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ : 30–06–2005.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಪಡೆದ ಭೂಮಾಲೀಕರು ಹೆಚ್ಚುವರಿ ಪರಿಹಾರ ಧನಕ್ಕಾಗಿ ರಾಮದುರ್ಗ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ದಾಖಲಿಸಿದ್ದ ಎಲ್.ಎ.ಸಿ ಪ್ರಕರಣ ಸಂಖ್ಯೆ : 79–82/07 ಮತ್ತು 84/07ರಲ್ಲಿ ಮಾನ್ಯ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನ ಪಾವತಿಸಲು ದಿನಾಂಕ : 24–04–2009ರ ಆದೇಶದಲ್ಲಿ ಪ್ರತಿ ಎಕರೆ ಜಮೀನಿಗೆ ರೂ. 1,80,000/–ಗಳನ್ನು ನಿಗದಿಪಡಿಸಿ ತೀರ್ಪು ನೀಡಿದೆ.

ಸಿವಿಲ್ ನ್ಯಾಯಾಲಯದ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಅಧಿಕಾರಿ–111(ಎಲ್‌ಎಸಿ) ಇವರು ಪತ್ರ ಸಂಖ್ಯೆ : ಆರ್‌ಡಿ 500 ಎಲ್‌ಸಿಬಿ 2010, ದಿನಾಂಕ : 13–10–2010 ಹಾಗೂ ಆರ್‌ಡಿ 1071 ಎಲ್‌ಸಿಬಿ 2010, ದಿನಾಂಕ : 05–02–2011 ರಂದು ಅಭಿಪ್ರಾಯ ನೀಡಿದೆ.

ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ :

| ಕ್ರ. ಸಂ. | ಎಲ್‌ಎಸಿ ಸಂಖ್ಯೆ | ಗ್ರಾಮ | ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 79/2007 | ಬಟಕುರ್ಕಿ | 523 | 2–36 | 1671021 |
| 2 | 80/2007 | ಚನ್ನಾಪೂರ | 9/1 | 0–26 | 374727 |
| 3 | 81/2007 | ಚನ್ನಾಪೂರ | 196/1,196/2 | 0–20 | 288321 |
| 4 | 82/2007 | ಚನ್ನಾಪೂರ | 194/1ಬಿ | 3–10 | 1872436 |
| 5 | 83/2007 | ಬಟಕುರ್ಕಿ | 536 | 2–26 | 1526811 |
| 6 | 84/2007 | ಬಟಕುರ್ಕಿ | 197,198 | 4–36 | 2822906 |
| ಒಟ್ಟು | | | | | **8556222–00** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ : ಸನೀಇ 03 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ : 30–03–2012**

ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ಬಟಕುರ್ಕಿ ಹಾಗೂ ಚನ್ನಾಪೂರ ಗ್ರಾಮದ ಹದ್ದಿಯಲ್ಲಿ ರಾಜನಾಳ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಸದರಿ ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕ ಹಾಕಿದ ಪರಿಹಾರ ಧನ ಮೊತ್ತ ರೂ. 85,56,222–00 ಗಳನ್ನು (ಎಂಭತ್ತೈದು ಲಕ್ಷದ ಐವತ್ತಾರು ಸಾವಿರದ ಇನ್ನೂರ ಇಪ್ಪತ್ತೆರಡು ರೂ.ಗಳು ಮಾತ್ರ) ಪಾವತಿಸಲು ಸರ್ಕಾರ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

4. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
5. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
6. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ಭರಿಸತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಅಧಿಕಾರ ಪ್ರತ್ಯಾಯೋಜನೆಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

ಪಿ.ಆರ್. 1119

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ಗೊಡಚಿ ಗ್ರಾಮದ ಹದ್ದಿಯಲ್ಲಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ಬೆಳೆ ನಷ್ಟ ಪರಿಹಾರ ನೀಡುವ ಬಗ್ಗೆ.

**ಓದಲಾಗಿದೆ :**
1. ಉಪ ವಿಭಾಗಾಧಿಕಾರಿಗಳು, ಬೈಲಹೊಮಗಲ ಇವರ ಆದೇಶ ಸಂಖ್ಯೆ : ಭೂಸ್ವಾವಿವಹಿ.ರಾ–93/ಎ/00–01, ದಿನಾಂಕ : 21–10–2011.
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಮರ ಇವರ ಪತ್ರ ಸಂಖ್ಯೆ : ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ/2011–12/6273, ದಿನಾಂಕ : 09–12–11.

**ಪ್ರಸ್ತಾವನೆ :**

ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕಿನ ಗೊಡಚಿ ಕೆರೆಯ ಮುಳುಗಡೆ ಪ್ರದೇಶದಲ್ಲಿ ಬರುವ ಗೊಡಚಿ ಗ್ರಾಮದ ಸವೆ ನಂಬರ್ 67/2+5+7, 68/1, 71 ಹಾಗೂ 47/1ರ 10–36 ಎಕರೆ ಖಾಸಗಿ ಜಮೀನನ್ನು ಸ್ವಾಧೀನಪಡಿಸಿಕೊಂಡಿದ್ದು, ಈ ಭೂಸ್ವಾಧೀನ ಪ್ರಕ್ರಿಯೆಯಲ್ಲಿ 4(1)ರ ಅಧಿಸೂಚನೆಯನ್ನು ದಿನಾಂಕ 11–05–2006ರಂದು ಮತ್ತು ಪರಿಹಾರ ಧನದ ಐತೀರ್ಪನ್ನು ದಿನಾಂಕ 21–10–11ರಂದು ಹೊರಡಿಸಲಾಗಿದೆ.

ಐತೀರ್ಪಿನಂತೆ ಪರಿಹಾರ ಪಡೆದ ಭೂಮಾಲೀಕರು ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಹೆಚ್ಚಿನ ಪರಿಹಾರಕ್ಕಾಗಿ ಸಿವಿಲ್ ನ್ಯಾಯಾಲಯ(ಹಿರಿಯ ವಿಭಾಗ) ಸವದತ್ತಿ ಇಲ್ಲಿ ಸಲ್ಲಿಸಿದ ಎಲ್.ಎ.ಸಿ. ಸಂಖ್ಯೆ : 110/08, 112/08, 115/08 ಮತ್ತು 135/08 ರಲ್ಲಿ ನ್ಯಾಯಾಲಯವು ಹೆಚ್ಚಿನ ಪರಿಹಾರಕ್ಕೆ ತೀರ್ಪು ನೀಡಿದ್ದು, ಈ ತೀರ್ಪಿನಂತೆ 4(1)ರ ಅಧಿಸೂಚನೆ ದಿನಾಂಕದಿಂದ ಲೆಕ್ಕ ಹಾಕಿದ ಬಡ್ಡಿಯೊಂದಿಗೆ ಪರಿಹಾರ ಧನವನ್ನು ನ್ಯಾಯಾಲಯದಲ್ಲಿ ಠೇವಣಿ ಮಾಡಲಾಗಿದೆ.

ಎಲ್.ಎ.ಸಿ ಪ್ರಕರಣಗಳಲ್ಲಿ ನ್ಯಾಯಾಲಯಕ್ಕೆ ದಾಖಲೆಗಳನ್ನು ಸಲ್ಲಿಸುವ ಸಂದರ್ಭದಲ್ಲಿ ಸ್ವಾಧೀನಕ್ಕೊಳಪಟ್ಟ ಜಮೀನುಗಳನ್ನು 1984ನೇ ಸಾಲಿನಲ್ಲಿ ಕಬ್ಜೆ ಪಡೆದಿರುವುದಾಗಿ ಕಾರ್ಯಪಾಲಕ ಅಭಿಯಂತರರು, ಸಣ್ಣ ನೀರಾವರಿ ಉಪ ವಿಭಾಗ ಬೆಳಗಾವಿ ಇವರು ನ್ಯಾಯಾಲಯಕ್ಕೆ ದಾಖಲೆ ಸಲ್ಲಿಸಿದ್ದರು. ಇದನ್ನು ಆಧರಿಸಿ ಜಮೀನಿನ ಕಬ್ಜೆ ದಿನಾಂಕದಿಂದ 4(1)ರ ಅಧಿಸೂಚನೆ ದಿನಾಂಕದವರೆಗೆ ಬೆಳೆನಷ್ಟ ಪರಿಹಾರ ಪಾವತಿಸಲು ಭೂಮಾಲೀಕರು ಸಲ್ಲಿಸಿದ್ದ ಅರ್ಜಿಯನ್ನು ಪರಿಶೀಲಿಸಿ, ಉಪ ವಿಭಾಗಾಧಿಕಾರಿ, ಬೈಲಹೊಂಗಲ ಇವರು ರೂ. 88,54,096–00ಗಳ ನಷ್ಟ ಪರಿಹಾರಕ್ಕೆ ಮೇಲೆ (1)ರಲ್ಲಿ ಓದಲಾದ ದಿನಾಂಕ : 21–10–2011ರಲ್ಲಿ ಆದೇಶ ಹೊರಡಿಸಿದ್ದಾರೆ. ಈ ಆದೇಶದಂತೆ ಭೂಮಾಲೀಕರಿಗೆ ನಷ್ಟ ಪರಿಹಾರ ಧನ ಪಾವತಿಸಲು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಹಣ ಬಿಡುಗಡೆ ಮಾಡುವಂತೆ ಮೇಲೆ (2)ರಲ್ಲಿ ಓದಲಾದ ದಿನಾಂಕ : 09–12–2011ರ ಪತ್ರದಲ್ಲಿ ಕೋರಿದ್ದಾರೆ.

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ : ಸನೀಇ 179 ಭೂಸ್ವಾಪ್ರ 2011, ಬೆಂಗಳೂರು, ದಿನಾಂಕ : 30–03–2012**

ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕಿನ ಗೊಡಚಿ ಗ್ರಾಮದ ಹದ್ದಿನಲ್ಲಿ ನಿರ್ಮಿಸಲಾದ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕೆ ಸ್ವಾಧೀನಪಡಿಸಿಕೊಂಡ ಗೊಡಚಿ ಗ್ರಾಮದ ಸ.ನಂ. 67/2+5+7, 68/1, 71 ಹಾಗೂ 47/1ರ 10–36 ಎಕರೆ ಜಮೀನಿಗೆ ಉಪವಿಭಾಗಾಧಿಕಾರಿ, ಬೈಲಹೊಂಗಲ ಇವರು ರಚಿಸಿರುವ ಐತೀರ್ಪಿನಂತೆ ರೂ. 88,54,096–00ಗಳ (ಎಂಭತ್ತೆಂಟು ಲಕ್ಷದ ಐವತ್ತನಾಲ್ಕು ಸಾವಿರದ ತೊಂಭತ್ತಾರು ರೂ.ಗಳು ಮಾತ್ರ) ಬೆಳೆನಷ್ಟ ಪರಿಹಾರ ಪಾವತಿಸಲು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ನೀಡಲು ಸರ್ಕಾರದ ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2 ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3 ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ಭರಿಸತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಪಿ.ಆರ್. 1120 ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ರಾಮನಗರ ಜಿಲ್ಲೆ ಮತ್ತು ತಾಲ್ಲೂಕು ಬಿಡದಿ ಹೋಬಳಿ ಮೇಡನಹಳ್ಳಿ ಹೊಸಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು ಪರಿಷ್ಕೃತ ಆದೇಶ.

**ಓದಲಾಗಿದೆ :**
1. ಸರ್ಕಾರದ ಆದೇಶ ಸಂಖ್ಯೆ : ಸನೀಇ 158 ಭೂಸ್ವಾಪ್ರ 2010, ದಿನಾಂಕ 30–03–2011.
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ಇವರ ಪತ್ರ ಸಂಖ್ಯೆ : ಮುಸದ/ಲೆಶಾಖೆ/ಲೆಸ–1/3/ಭೂಸ್ವಾಧೀನ/ಅನುದಾನ/2011–12/143, ದಿನಾಂಕ : 13–01–2012.

**ಪ್ರಸ್ತಾವನೆ :**

ರಾಮನಗರ ಜಿಲ್ಲೆ ಮತ್ತು ತಾಲ್ಲೂಕು ಬಿಡದಿ ಹೋಬಳಿ ಮೇಡನಹಳ್ಳಿ ಹೊಸಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ರಾಮನಗರ ಸಿವಿಲ್ ನ್ಯಾಯಾಲಯವು (ಹಿರಿಯ ಶ್ರೇಣಿ) ಭೂಸ್ವಾಧೀನದ ಎಲ್.ಎ.ಸಿ. ಪ್ರಕರಣದಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಮೇಲೆ (1)ರಲ್ಲಿ ಓದಲಾದ ದಿನಾಂಕ : 30–03–2011ರ ಸರ್ಕಾರದ ಆದೇಶದಲ್ಲಿ ಅನುಮೋದನೆ ನೀಡಲಾಗಿದೆ.

ಸರ್ಕಾರದ ಆದೇಶದಲ್ಲಿ ಹೆಚ್ಚಿನ ಪರಿಹಾರ ಧನಕ್ಕೆ ಮಂಜೂರಾತಿ ನೀಡಿದ ಪ್ರಕರಣದ ವಿವರ ಕೆಳಕಂಡಂತಿದೆ :

| ಕ್ರ. ಸಂ. | ಎಲ್‌ಎಸಿ ಸಂಖ್ಯೆ | ಬಾನಂದೂರು ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 27/81 | 108/21 | 0–17 | 56708 |
| | | 108/20 | 1–03 | 35508 |
| | | 109 | 1–00 | 5506 |
| | | 109 | 1–01 | 37622 |
| | **ಒಟ್ಟು** | | | **135344** |

ಮೇಲ್ಕಂಡ ಹೆಚ್ಚಿನ ಪರಿಹಾರ ಮೊತ್ತವನ್ನು 2010–11ನೇ ಸಾಲಿನ ಆಯವ್ಯಯದ ಲೆಕ್ಕ ಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ಭರಿಸುವಂತೆ ಸದರಿ ಆದೇಶದಲ್ಲಿ ಸೂಚಿಸಲಾಗಿತ್ತು. ಸದರಿ ಆದೇಶದ ಪ್ರತಿಯು ಮುಖ್ಯ ಇಂಜಿನಿಯರ್‌ರವರಿಗೆ ತಲುಪಿರುವುದಿಲ್ಲವಾದುದರಿಂದ, ಭೂಮಾಲೀಕರಿಗೆ ಹಣ ಪಾವತಿಯಾಗಿರುವುದಿಲ್ಲವೆಂದು ಮುಖ್ಯ ಇಂಜಿನಿಯರ್‌ರವರು ಮೇಲೆ (2)ರಲ್ಲಿ ಓದಲಾದ ಪತ್ರದಲ್ಲಿ ತಿಳಿಸಿದ್ದಾರೆ. ಆದ್ದರಿಂದ, 2011–12ನೇ ಸಾಲಿನಲ್ಲಿ ಈ ಶೀರ್ಷಿಕೆಯಡಿ ಒದಗಿಸಿರುವ ಪೂರಕ ಅನುದಾನದಲ್ಲಿ ಭರಿಸಲು ದಿನಾಂಕ : 30–03–2011ರ ಆದೇಶವನ್ನು ಪರಿಷ್ಕರಿಸಿ ಈ ಕೆಳಕಂಡಂತೆ ಆದೇಶ ಹೊರಡಿಸಲು ಸರ್ಕಾರವು ನಿರ್ಧರಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 25 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ : 30–03–2012**

ದಿನಾಂಕ 30–03–2011ರಂದು ಹೊರಡಿಸಲಾದ ಸರ್ಕಾರದ ಆದೇಶ ಸಂಖ್ಯೆ : ಸನೀಇ 158 ಭೂಸ್ವಾಪ್ರ 2010ರಲ್ಲಿ ಪರಿಹಾರ ಮೊತ್ತ ರೂ. 1,35,344–00ಗಳಿಗೆ ಅನುಮೋದನೆ ನೀಡಲಾಗಿದ್ದು, ಸದರಿ ಮೊತ್ತವನ್ನು ಉಪಯೋಗಿಸದೇ ಇದ್ದ ಹಿನ್ನೆಲೆಯಲ್ಲಿ ದಿನಾಂಕ : 30–03–2011ರ ಆದೇಶವನ್ನು ಹಿಂಪಡೆದು, ಪರಿಷ್ಕೃತ ಆದೇಶವನ್ನು ಹೊರಡಿಸುವ ಬಗ್ಗೆ ಪರಿಶೀಲಿಸಿ ಪ್ರಸ್ತಾವನೆಯಲ್ಲಿ ತಿಳಿಸಿರುವ ಎಲ್.ಎ.ಸಿ. ಪ್ರಕರಣಕ್ಕೆ ರೂ. 1,35,344–00ಗಳ (ಒಂದು ಲಕ್ಷದ ಮುವತ್ತೈದು ಸಾವಿರದ ಮುನ್ನೂರ ನಲವತ್ತ ನಾಲ್ಕು ರೂ.ಗಳು ಮಾತ್ರ) ಹೆಚ್ಚಿನ ಪರಿಹಾರ ಧನ ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ಭರಿಸತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಅಧಿಕಾರ ಪ್ರತ್ಯಾಯೋಜನೆಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಪಿ.ಆರ್. 1121 ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೆಂಗಳೂರು ಗ್ರಾಮಾಂತರ ಜಿಲ್ಲೆ, ದೊಡ್ಡಬಳ್ಳಾಪುರ ತಾಲ್ಲೂಕು, ಮೂಡ್ಲಕಾಳೇನಹಳ್ಳಿ ಕೆರೆ ಸಣ್ಣ ನೀರಾವರಿ ಕೆರೆ ನಿರ್ಮಾಣ ಕಾಮಗಾರಿಗಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ನ್ಯಾಯಾಲಯದ ಆದೇಶಾನುಸಾರ ಹೆಚ್ಚುವರಿ ಪರಿಹಾರ ಧನ ಪಾವತಿಸುವ ಬಗ್ಗೆ.

**ಓದಲಾಗಿದೆ :**

1. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ಇವರ ದಿನಾಂಕ : 07–12–2009 ರಂದು ಕೊನೆಗೊಂಡ ಪತ್ರ ಸಂಖ್ಯೆ: ಮುಸದ/ಲೆಶಾ/ಲೆಸ–1/ಭೂಸ್ವಾಧೀನ/3/2009–10/3457.
2. ಉಪ ವಿಭಾಗಾಧಿಕಾರಿಗಳು, ದೊಡ್ಡಬಳ್ಳಾಪುರ ಉಪ ವಿಭಾಗ, ಇವರ ದಿನಾಂಕ 11–11–2011 ರಂದು ಅಂತ್ಯಗೊಂಡ ಪತ್ರ ಸಂಖ್ಯೆ : ಎಲ್‌ಎಕ್ಯೂ/ಎಸ್.ಆರ್.–1/1990–91.
3. ಸರ್ಕಾರದ ಆದೇಶ ಸಂಖ್ಯೆ : ಸನೀಇ 123 ಭೂಸ್ವಾಪ್ರ 2004, ದಿನಾಂಕ : 27–07–2006.

**ಪ್ರಸ್ತಾವನೆ :**

ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ಇವರು ಮೇಲೆ ಓದಲಾದ ಪತ್ರದಲ್ಲಿ ಬೆಂಗಳೂರು ಗ್ರಾಮಾಂತರ ಜಿಲ್ಲೆ, ದೊಡ್ಡಬಳ್ಳಾಪುರ ತಾಲ್ಲೂಕು ಮೂಡ್ಲಕಾಳೇನಹಳ್ಳಿ ಕೆರೆ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಮೂಡ್ಲಕಾಳೇನಹಳ್ಳಿ ಗ್ರಾಮದ

ಜಮೀನುಗಳಿಗೆ ನ್ಯಾಯಾಲಯವು ನೀಡಿರುವ ತೀರ್ಪಿನನುಸಾರ ಹೆಚ್ಚುವರಿ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿರುತ್ತಾರೆ. ಹೆಚ್ಚುವರಿ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನ ಪ್ರಕ್ರಿಯೆ ವಿವರಗಳು ಈ ಕೆಳಕಂಡಂತಿವೆ.

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 15-08-1999.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 11(ಎ)ರಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ : 15-03-1994.
- ಜಮೀನಿನ ಕಬ್ಜೆ ಪಡೆದ ದಿನಾಂಕ : 20-01-1980.

ಭೂಸ್ವಾಧೀನಕ್ಕೊಳಪಟ್ಟ ಮೂಡ್ಲಕಾಳೇನಹಳ್ಳಿ ಗ್ರಾಮದ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳು ರಚಿಸಿದ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು ಇನ್ನೂ ಹೆಚ್ಚಿನ ಪರಿಹಾರ ನೀಡುವಂತೆ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಸಿವಿಲ್ ನ್ಯಾಯಾಲಯದಲ್ಲಿ ಭೂಸ್ವಾಧೀನ ಪ್ರಕರಣ ಸಂಖ್ಯೆ : 113/96ನ್ನು ದಾಖಲಿಸಿದ್ದು, ಈ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಪಾವತಿಸುವಂತೆ ಹಾಗೂ ಹೆಚ್ಚುವರಿ ಪರಿಹಾರಧನಕ್ಕೆ ಬಡ್ಡಿಯನ್ನು ಕಬ್ಜೆ ದಿನಾಂಕದಿಂದ ನೀಡುವಂತೆ ಆದೇಶಿಸಿ, ದಿನಾಂಕ : 20-11-2000 ದಂದು ತೀರ್ಪು ನೀಡಿದೆ. ಈ ಭೂಸ್ವಾಧೀನ ಪ್ರಕರಣದಲ್ಲಿ 4(1)ರ ಅಧಿಸೂಚನೆಗಿಂತ ಮೊದಲು ಭೂಮಿಯನ್ನು ಕಬ್ಜೆ ಪಡೆದಿದ್ದು, ಸದರಿ ದಿನಾಂಕದಿಂದ ಪರಿಹಾರ ಧನದ ಮೇಲೆ ಬಡ್ಡಿ ಲೆಕ್ಕಹಾಕಲಾಗಿದ್ದು, ಭೂಸ್ವಾಧೀನ ತಿದ್ದುಪಡಿ ಕಾಯ್ದೆಯನುಸಾರ 4(1)ರ ಅಧಿಸೂಚನೆ ದಿನಾಂಕದಿಂದ ಮಾತ್ರ ಪರಿಗಣಿಸಿ ಅದರಂತೆ ರೂ. 16,65,566-00 ಗಳನ್ನು ಪಾವತಿಸಲು ಮೇಲೆ ಓದಲಾದ (3)ರ ಆದೇಶದಲ್ಲಿ ಮಂಜೂರಾತಿ ನೀಡಲಾಗಿದೆ. ಅದರಂತೆ ಈ ಮೊತ್ತವನ್ನು ನ್ಯಾಯಾಲಯದಲ್ಲಿ ಠೇವಣಿ ಮಾಡಲಾಗಿದ್ದು, ಪ್ರಕರಣವನ್ನು ನ್ಯಾಯಾಲಯವು ಮುಕ್ತಾಯಗೊಳಿಸದೆ ಡಿಕ್ರಿ ಆದೇಶದಂತೆ ಪೂರ್ಣ ಮೊತ್ತವನ್ನು ಪಾವತಿಸಲು ಜಪ್ತಿ ವಾರೆಂಟ್ ಜಾರಿಗೊಳಿಸಿದ ಕಾರಣ, ಮೇಲೆ ಓದಲಾದ (2)ರ ಪತ್ರದಲ್ಲಿ ಉಪವಿಭಾಗಾಧಿಕಾರಿಗಳು, ದೊಡ್ಡಬಳ್ಳಾಪುರ ಇವರು ಜಪ್ತಿ ಆದೇಶ ಜಾರಿಯಾದ ಕಾರಣ ಸದರಿ ಮೊತ್ತವನ್ನು ಬಿಡುಗಡೆ ಮಾಡುವಂತೆ ಕೋರಿರುತ್ತಾರೆ. ಈ ಬಗ್ಗೆ ಕಾನೂನು ಇಲಾಖೆಯ ಅಭಿಪ್ರಾಯವನ್ನು ಪಡೆಯಲಾಗಿದೆ.

ಸಿವಿಲ್ ನ್ಯಾಯಾಲಯವು ಹೆಚ್ಚುವರಿ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣದ ವಿವರ ಈ ಕೆಳಕಂಡಂತಿದೆ :

| ಕ್ರ. ಸಂ. | ಎಲ್ಎಸಿ ಸಂಖ್ಯೆ | ಮೂಡ್ಲಕಾಳೇನಹಳ್ಳಿ ಗ್ರಾಮದ ಸರ್ವೆ ನಂಬರ್ | ವಿಸ್ತೀರ್ಣ ಎ-ಗುಂ |
|---|---|---|---|
| 1 | 113/96 | 46 | 1-20 |
| 2 | 113/96 | 8 | 1-00 |
| 3 | 113/96 | 63/3 | 3-12 |

- **ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.**

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ, ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 31 ಭೂಸ್ವಾಪ್ರ 2008, ಬೆಂಗಳೂರು, ದಿನಾಂಕ : 31-03-2012**

ಬೆಂಗಳೂರು ಗ್ರಾಮಾಂತರ ಜಿಲ್ಲೆ, ದೊಡ್ಡಬಳ್ಳಾಪುರ ತಾಲ್ಲೂಕು ಮೂಡ್ಲಕಾಳೇನಹಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಮೂಡ್ಲಕಾಳೇನಹಳ್ಳಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನಿಗೆ ನ್ಯಾಯಾಲಯವು ನೀಡಿದ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕ ಹಾಕಿದ ಪರಿಹಾರ ಮೊತ್ತ ರೂ. 20,47,714-00 ಗಳನ್ನು (ಇಪ್ಪತ್ತು ಲಕ್ಷದ ನಲವತ್ತೇಳು ಸಾವಿರದ ಏಳು ನೂರ ಹದಿನಾಲ್ಕು ರೂ.ಗಳು ಮಾತ್ರ) ಗಳನ್ನು ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2011-12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702-0-800-1-00-ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು-ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ಭರಿಸತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20-10-2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಪಿ.ಆರ್. 1122 ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬಿಜಾಪುರ ಜಿಲ್ಲೆ, ಬ.ಬಾಗೇವಾಡಿ ತಾಲ್ಲೂಕು ಹೂವಿನ ಹಿಪ್ಪರಗಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಉಪ ವಿಭಾಗಾಧಿಕಾರಿಗಳು ಭೂಸ್ವಾಧೀನ ಕಾಯ್ದೆ ಕಲಂ 28(ಎ)ರ ಐತೀರ್ಪಿನಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ :09-12-2011ರ ಪತ್ರ ಸಂಖ್ಯೆ : ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011-12/6272.

**ಪ್ರಸ್ತಾವನೆ :**

ಮೇಲೆ ಓದಲಾದ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ದಿನಾಂಕ : 09–12–2011ರ ಪತ್ರದಲ್ಲಿ ಬಿಜಾಪುರ ಜಿಲ್ಲೆ, ಬ.ಬಾಗೇವಾಡಿ ತಾಲ್ಲೂಕು ಹೂವಿನ ಹಿಪ್ಪರಗಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಸಂಕನಾಳ ಮತ್ತು ಹೂವಿನ ಹಿಪ್ಪರಗಿ ಗ್ರಾಮದ ಜಮೀನುಗಳಿಗೆ ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಡಿ ಪ್ರಕಾರ ಉಪ ವಿಭಾಗಾಧಿಕಾರಿಗಳು, ಬಿಜಾಪುರ ಇವರು ಹೊರಡಿಸಿರುವ ಐತೀರ್ಪಿನಂತೆ ಹೆಚ್ಚಿನ ಪರಿಹಾರ ಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಈ ಕೆರೆಯ ಮೂಲ ಭೂಸ್ವಾಧೀನ ಪ್ರಕ್ರಿಯೆಯ ವಿವರಗಳು ಕೆಳಕಂಡಂತಿದೆ :

– ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 20–05–1986.

– ಉಪ ವಿಭಾಗಾಧಿಕಾರಿಗಳ ಐತೀರ್ಪಿನ ದಿನಾಂಕ : 19–03–1987.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಬ.ಬಾಗೇವಾಡಿ ಸಿವಿಲ್ ನ್ಯಾಯಾಲಯ (ಹಿರಿಯ ವಿಭಾಗ) ದಲ್ಲಿ ದಾಖಲಿಸಿದ್ದ ಎಲ್.ಎ.ಸಿ. ಸಂಖ್ಯೆ : 7/05 ಮತ್ತು 8/05ರ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ದಿನಾಂಕ : 14–12–2007ರಂದು ನೀಡಿರುವ ಆದೇಶದಲ್ಲಿ ಪ್ರತಿ ಎಕರೆಗೆ ರೂ. 40,000/–ಗಳನ್ನು ನಿಗದಿಪಡಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶವು ಪತ್ರ ಸಂಖ್ಯೆ : ಆರ್‌ಡಿ 1131 ಎಲ್‌ಸಿಬಿ 2008, ದಿನಾಂಕ : 16–04–2009ರಲ್ಲಿ ಅಭಿಪ್ರಾಯ ನೀಡಿದೆ.

ಸಿವಿಲ್ ನ್ಯಾಯಾಲಯದ ತೀರ್ಪನ್ನು ಆಧರಿಸಿ ಭೂಸ್ವಾಧೀನದಲ್ಲಿ ಸೇರಿದ್ದ ಇತರೆ ಈ ಕೆಳಕಂಡ ಸ.ನಂ.ಗಳ ಭೂಮಾಲೀಕರು ಹೆಚ್ಚಿನ ಪರಿಹಾರ ಕೋರಿ ಸಲ್ಲಿಸಿದ ಅರ್ಜಿಯ ಮೇರೆಗೆ ಉಪವಿಭಾಗಾಧಿಕಾರಿ ಹಾಗೂ ಭೂಸ್ವಾಧೀನಾಧಿಕಾರಿಗಳು, ಬಿಜಾಪುರ ಇವರು ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಡಿ ದಿನಾಂಕ : 10–01–2011 ರಂದು ಐತೀರ್ಪನ್ನು ರಚಿಸಿರುತ್ತಾರೆ.

| ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಡಿ ಐತೀರ್ಪಿನ ಸಂಖ್ಯೆ ಎಲ್ಎಕ್ಯೂ ಎಸ್.ಆರ್.–2/85–86(ಅ), ದಿನಾಂಕ : 10–01–2011 | | | | |
|---|---|---|---|---|
| ಕ್ರ. ಸಂ. | ಸ.ನಂ. | ವಿಸ್ತೀರ್ಣ ಎ–ಗುಂ | ಗ್ರಾಮ | ಪರಿಹಾರ ಮೊತ್ತ ರೂ.ಗಳಲ್ಲಿ |
| 1 | 105/1–4 | 2–19 | ಹೂವಿನ ಹಿಪ್ಪರಗಿ | 548613 |
| 2 | 96/1 | 7–20 | ಹೂವಿನ ಹಿಪ್ಪರಗಿ | 1451357 |
| 3 | 104 | 3–14 | ಹೂವಿನ ಹಿಪ್ಪರಗಿ | 746496 |
| 4 | 96/2ಸಿ | 1–20 | ಹೂವಿನ ಹಿಪ್ಪರಗಿ | 290271 |
| 5 | 96/2ಬಿ | 4–00 | ಹೂವಿನ ಹಿಪ್ಪರಗಿ | 774057 |
| 6 | 97 | 0–36 | ಹೂವಿನ ಹಿಪ್ಪರಗಿ | 192107 |
| 7 | 509/1–3 | 0–28 | ಹೂವಿನ ಹಿಪ್ಪರಗಿ | 157831 |
| 8 | 396 | 0–05 | ಹೂವಿನ ಹಿಪ್ಪರಗಿ | 28184 |
| 9 | 95/2 | 8–24 | ಹೂವಿನ ಹಿಪ್ಪರಗಿ | 1664223 |
| 10 | 103 | 2–08 | ಹೂವಿನ ಹಿಪ್ಪರಗಿ | 487656 |
| 11 | 99 | 2–00 | ಹೂವಿನ ಹಿಪ್ಪರಗಿ | 443324 |
| | **ಒಟ್ಟು** | | | **6784119** |

ವಿಷಯವನ್ನು ಪರಿಶೀಲಿಸಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ : ಸನೀಇ 12 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ : 30–03–2012**

ಬಿಜಾಪುರ ಜಿಲ್ಲೆ, ಬ.ಬಾಗೇವಾಡಿ ತಾಲ್ಲೂಕು ಹೂವಿನ ಹಿಪ್ಪರಗಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಸಂಕನಾಳ ಮತ್ತು ಹೂವಿನ ಹಿಪ್ಪರಗಿ ಗ್ರಾಮದ ಜಮೀನುಗಳಿಗೆ ಭೂಸ್ವಾಧೀನ ಕಾಯ್ದೆ ಕಲಂ 28(ಎ)ರ ಪ್ರಕಾರ ಉಪ ವಿಭಾಗಾಧಿಕಾರಿಗಳು, ಬಿಜಾಪುರ ಇವರು ಹೊರಡಿಸಿರುವ ಐತೀರ್ಪಿನಂತೆ ಪರಿಹಾರ ಧನದ ಮೊತ್ತ ರೂ. 67,84,119–00ಗಳನ್ನು (ಅರವತ್ತೇಳು ಲಕ್ಷದ ಎಂಭತ್ತನಾಲ್ಕು ಸಾವಿರದ ಒಂದು ನೂರ ಹತ್ತೊಂಭತ್ತು ರೂ.ಗಳು ಮಾತ್ರ) ಪ್ರಸ್ತಾವನೆಯಲ್ಲಿ ತಿಳಿಸಿರುವ ಸ.ನಂ.ಗಳಿಗೆ ಪಾವತಿಸಲು ಸರ್ಕಾರವು ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 67,84,119/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2010 ದಿನಾಂಕ : 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

ಪಿ.ಆರ್. 1123

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬಿಜಾಪುರ ಜಿಲ್ಲೆ, ಸಿಂಧಗಿ ತಾಲ್ಲೂಕು ಪಡಗಾನೂರ ಸಣ್ಣ, ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪಾವತಿಸುವ ಕುರಿತು.

**ಓದಲಾಗಿದೆ :** 1. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ: 30–12–2011ರ ಪತ್ರ ಸಂಖ್ಯೆ: ಮುಇಂ/ಸನೀ(ಉ)ವ/ಭೂಸ್ವಾಪ್ರ/2011–12/6664.

**ಪ್ರಸ್ತಾವನೆ :**

ಬಿಜಾಪುರ ಜಿಲ್ಲೆ, ಸಿಂಧಗಿ ತಾಲ್ಲೂಕು ಪಡಗಾನೂರ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಶಿವಣಗಿ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ಪತ್ರದಲ್ಲಿ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 20–11–1997
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ: 19–08–2000.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಬಿಜಾಪುರ 2ನೇ ಸಿವಿಲ್ ಜಡ್ಜ್ (ಹಿರಿಯ ವಿಭಾಗ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣವನ್ನು ದಾಖಲಿಸಿದ್ದು, ನ್ಯಾಯಾಲಯವು ಪ್ರತಿ ಎಕರೆ ರೂ. 37,000/– ಗಳನ್ನು ನಿಗದಿಪಡಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶವು ಅಭಿಪ್ರಾಯ ನೀಡಿದೆ. ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ.

| ಕ್ರ.ಸಂ. | ಎಲ್.ಎ.ಸಿ ಸಂಖ್ಯೆ | ಶಿವಣಗಿ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ. ಗಳಲ್ಲಿ) |
|---|---|---|---|---|
| 1. | 271/02 | 432 | 4–18 | 3,63,418–00 |
| | **ಒಟ್ಟು** | | | **3,63,418–00** |

- ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 16 ಭೂಸ್ವಾಪ್ರ 2011 ಬೆಂಗಳೂರು, ದಿನಾಂಕ: 31ನೇ ಮಾರ್ಚ್ 2012**

ಬಿಜಾಪುರ ಜಿಲ್ಲೆ ಸಿಂಧಗಿ ತಾಲ್ಲೂಕು ಪಡಗಾನರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಶಿವಣಗಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ. 3,63,418–00 ಗಳನ್ನು (ಮೂರು ಲಕ್ಷದ ಅರವತ್ತೂರು ಸಾವಿರದ ನಾನೂರ ಹದಿನೆಂಟು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು. ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2010–11ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00 ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 3,63,418/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ: 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ.ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಪಿಆರ್ ನಂ. 1124 ಜಲಸಂಪನ್ಮೂಲ ಇಲಾಖೆ. (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬಿಜಾಪುರ ಜಿಲ್ಲೆ, ಮುದ್ದೆಬಿಹಾಳ ತಾಲ್ಲೂಕು ಮಾದಿನಾಳ ಗ್ರಾಮದ ವಸರು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಧನ ಪಾವತಿಸುವ ಕುರಿತು.

**ಓದಲಾಗಿದೆ :** 1. ಸರ್ಕಾರದ ಆದೇಶ ಸಂಖ್ಯೆ: ಸನೀಇ 120 ಭೂಸ್ವಾಪ್ರ 2011, ದಿನಾಂಕ : 28–10–2011.

2. ಸರ್ಕಾರದ ತಿದ್ದುಪಡಿ ಆದೇಶ ಸಂಖ್ಯೆ: ಸನೀಇ 120 ಭೂಸ್ವಾಪ್ರ 2011, ದಿನಾಂಕ: 04–01–2012.

**ಪ್ರಸ್ತಾವನೆ :**

ಬಿಜಾಪುರ ಜಿಲ್ಲೆ, ಮುದ್ದೆಬಿಹಾಳ ತಾಲ್ಲೂಕಿನ ಮಾದಿನಾಳ ಗ್ರಾಮದ ವಸರು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಮುದ್ದೇಬಿಹಾಳ ಸಿವಿಲ್ ನ್ಯಾಯಾಲಯವು (ಹಿರಿಯ ಶ್ರೇಣಿ) ಭೂಸ್ವಾಧೀನದ ಎಲ್.ಎ.ಸಿ. ಪ್ರಕರಣದಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು 7 ಎಲ್.ಎ.ಸಿ. ಪ್ರಕರಣಗಳಿಗೆ ಮೇಲೆ (1)ರಲ್ಲಿ ಓದಲಾದ ಸರ್ಕಾರದ ಆದೇಶದಲ್ಲಿ ಅನುಮೋದನೆ ನೀಡಲಾಗಿದೆ. ನಂತರ ಮೇಲೆ (2)ರಲ್ಲಿ ಓದಲಾದ ತಿದ್ದುಪಡಿ ಆದೇಶದಲ್ಲಿ ಎಲ್.ಎ.ಸಿ. ಸಂಖ್ಯೆ: 21/04ನ್ನು ಹೊರತುಪಡಿಸಿ ಇನ್ನುಳಿದ 6 ಎಲ್.ಎ.ಸಿ ಪ್ರಕರಣಗಳಿಗೆ ಹಣ ಪಾವತಿಸಲು ಅನುಮೋದನೆ ನೀಡಿದೆ. ಪ್ರಸ್ತುತ ಬಾಕಿ ಉಳಿದ ಎಲ್.ಎ.ಸಿ. ಪ್ರಕರಣ ಸಂಖ್ಯೆ: 21/04, ಸ.ನಂ. 100/1ರ 0–28 ಎಕರೆ ವಿಸ್ತೀರ್ಣದ ಜಮೀನಿಗೆ ಪರಿಹಾರ ಧನ ಪಾವತಿಸುವ ಬಗ್ಗೆ ಪರಿಶೀಲಿಸಿ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 120 ಭೂಸ್ವಾಪ್ರ 2011 ಬೆಂಗಳೂರು, ದಿನಾಂಕ : 30ನೇ ಮಾರ್ಚ್ 2012**

ಬಿಜಾಪುರ ಜಿಲ್ಲೆ ಮುದ್ದೇಬಿಹಾಳ ತಾಲ್ಲೂಕಿನ ಮಾದಿನಾಳ ಗ್ರಾಮದ ವಸರು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಮೇಲ್ಕಂಡ ಸರ್ವೆ ನಂಬರ್ ಜಮೀನಿಗೆ ಮುದ್ದೇಬಿಹಾಳ ಸಿವಿಲ್ ನ್ಯಾಯಾಲಯವು (ಹಿರಿಯ ಶ್ರೇಣಿ) ಎಲ್.ಎ.ಸಿ. ಸಂಖ್ಯೆ: 21/04ರಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯನುಸಾರ ರೂ. 1,97,49–00ಗಳ (ಒಂದು ಲಕ್ಷದ ತೊಂಭತ್ತೇಳು ಸಾವಿರದ ಆರನೂರ ನಲವತ್ತೊಂಭತ್ತು ರೂ.ಗಳು ಮಾತ್ರ) ಹೆಚ್ಚಿನ ಪರಿಹಾರ ಧನ ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು. ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00 ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 1,97,649/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ : 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಅಧಿಕಾರ ಪ್ರತ್ಯಾಯೋಜನೆಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ.ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಪಿಆರ್ ನಂ. 1125 ಜಲಸಂಪನ್ಮೂಲ ಇಲಾಖೆ. (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬಿಜಾಪುರ ಜಿಲ್ಲೆ, ಬ. ಬಾಗೇವಾಡಿ ತಾಲ್ಲೂಕು ಮುಕುರ್ತಿಹಾಳ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಸಂಕನಾಳ ಗ್ರಾಮದ ಜಮೀನುಗಳಿಗೆ ಉಪ ವಿಭಾಗಾಧಿಕಾರಿಗಳು ಭೂಸ್ವಾಧೀನ ಕಾಯ್ದೆ ಕಲಂ 28(ಎ)ರ ಐತೀರ್ಪಿನಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ :** 1. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ: 21-09-2011ರ ಪತ್ರ ಸಂಖ್ಯೆ: ಮುಇಂ/ಸನೀ(ಉ)ವ/ಭೂಸ್ವಾಪ್ರ/2011-12/4888.

**ಪ್ರಸ್ತಾವನೆ :**

ಮೇಲೆ ಓದಲಾದ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ದಿನಾಂಕ:21-09-2011ರ ಪತ್ರದಲ್ಲಿ ಬಿಜಾಪುರ ಜಿಲ್ಲೆ, ಬ.ಬಾಗೇವಾಡಿ ತಾಲ್ಲೂಕು ಮುಕುರ್ತಿಹಾಳ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಸಂಕನಾಳ ಗ್ರಾಮದ ಜಮೀನುಗಳಿಗೆ ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಡಿ ಪ್ರಕಾರ ಉಪ ವಿಭಾಗಾಧಿಕಾರಿಗಳು, ಬಿಜಾಪುರ ಇವರು ಹೊರಡಿಸಿರುವ ಐತೀರ್ಪಿನಂತೆ ಹೆಚ್ಚಿನ ಪರಿಹಾರ ಧನ ಪಾವತಿಸಲು ರೂ. 24,46,843-00ಗಳನ್ನು ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಈ ಕೆರೆಯ ಮೂಲ ಭೂಸ್ವಾಧೀನ ಪ್ರಕ್ರಿಯೆಯ ವಿವರಗಳ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 01-05-1986.
- ಉಪ ವಿಭಾಗಾಧಿಕಾರಿಗಳ ಐತೀರ್ಪಿನ ದಿನಾಂಕ: 10-08-1987.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಬ.ಬಾಗೇವಾಡಿ ಸಿವಿಲ್ ನ್ಯಾಯಾಲಯ (ಹಿರಿಯ ವಿಭಾಗ)ದಲ್ಲಿ ದಾಖಲಿಸಿದ್ದ ಎಲ್.ಎ.ಸಿ. ಸಂಖ್ಯೆ: 69/03ರ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ದಿನಾಂಕ: 20-03-2006ರಂದು ನೀಡಿರುವ ಆದೇಶದಲ್ಲಿ ಪ್ರತಿ ಎಕರೆಗೆ ರೂ. 53,300/-ಗಳನ್ನು ನಿಗದಿಪಡಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು ಇಲಾಖೆಯ ಪತ್ರ ಸಂಖ್ಯೆ: ಲಾ 1846 ಎಲ್‌ಬಿಎಸ್ 2006, ದಿನಾಂಕ: 22-08-2006ರಲ್ಲಿ ಅಭಿಪ್ರಾಯ ನೀಡಿದೆ.

ಸಿವಿಲ್ ನ್ಯಾಯಾಲಯದ ತೀರ್ಪನ್ನು ಆಧರಿಸಿ ಭೂಸ್ವಾದೀನದಲ್ಲಿ ಸೇರಿದ್ದ ಇತರೆ ಈ ಕೆಳಕಂಡ ಸ.ನಂ.ಗಳ ಭೂಮಾಲೀಕರು ಹೆಚ್ಚಿನ ಪರಿಹಾರ ಕೋರಿ ಸಲ್ಲಿಸಿದ ಅರ್ಜಿಯ ಮೇರೆಗೆ ಉಪವಿಭಾಗಾಧಿಕಾರಿ ಹಾಗೂ ಭೂಸ್ವಾದೀನಾಧಿಕಾರಿಗಳು, ಬಿಜಾಪುರ ಇವರು ಭೂಸ್ವಾದೀನ ಕಾಯ್ದೆ ಕಲಂ 28(ಎ)ರಡಿ ದಿನಾಂಕ: 29-09-2010ರಂದು ಐತೀರ್ಪನ್ನು ರಚಿಸಿರುತ್ತಾರೆ.

| ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಡಿ ಐತೀರ್ಪಿನ ಸಂಖ್ಯೆ ಎಲ್‌ಎಕ್ಯೂಎಸ್‌ಆರ್-823(ಅ)28(ಎ), ದಿನಾಂಕ: 29-09-10 | | | | |
|---|---|---|---|---|
| ಕ್ರ.ಸಂ. | ಸ.ನಂ. | ವಿಸ್ತೀರ್ಣ ಎ-ಗುಂ | ಗ್ರಾಮ | ಪರಿಹಾರ ಮೊತ್ತ (ರೂ.ಗಳಲ್ಲಿ) |
| 1 | 31 | 0-21 | ಮುಕುರ್ತಿಹಾಳ | 177351 |
| 2 | 34 | 2-25 | ಮುಕುರ್ತಿಹಾಳ | 886753 |
| 3 | 32 | 0-07 | ಮುಕುರ್ತಿಹಾಳ | 60168 |
| 4 | 153 | 0-14 | ಮುಕುರ್ತಿಹಾಳ | 119869 |
| 5 | 64 | 0-01 | ಮುಕುರ್ತಿಹಾಳ | 8595 |
| 6 | 113 | 0-01 | ಮುಕುರ್ತಿಹಾಳ | 8595 |
| 7 | 100 | 0-1.5 | ಮುಕುರ್ತಿಹಾಳ | 12668 |
| 8 | 102 | 0-08 | ಮುಕುರ್ತಿಹಾಳ | 68764 |
| 9 | 107 | 0-22 | ಮುಕುರ್ತಿಹಾಳ | 182124 |
| 10 | 115 | 0-03 | ಮುಕುರ್ತಿಹಾಳ | 120337 |
| 11 | 51 | 0-14 | ಮುಕುರ್ತಿಹಾಳ | 25686 |
| 12 | 71 | 0-03 | ಮುಕುರ್ತಿಹಾಳ | 25686 |
| 13 | 61 | 0-10 | ಮುಕುರ್ತಿಹಾಳ | 85955 |
| 14 | 58/1 | 1-30 | ಮುಕುರ್ತಿಹಾಳ | 601685 |
| 15 | 112 | 0-0.5 | ಮುಕುರ್ತಿಹಾಳ | 4298 |
| | **ಒಟ್ಟು** | | | **2388534** |

ವಿಷಯವನ್ನು ಪರಿಶೀಲಿಸಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 143 ಭೂಸ್ವಾಪ್ರ 2011 ಬೆಂಗಳೂರು, ದಿನಾಂಕ: 30ನೇ ಮಾರ್ಚ್ 2012**

ಬಿಜಾಪುರ ಜಿಲ್ಲೆ ಬ.ಬಾಗೇವಾಡಿ ತಾಲ್ಲೂಕು ಮುಕರ್ತಿಹಾಳ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಮುಕರ್ತಿಹಾಳ ಗ್ರಾಮದ ಜಮೀನುಗಳಿಗೆ ಭೂಸ್ವಾಧೀನ ಕಾಯ್ದೆ ಕಲಂ 28(ಎ) ಪ್ರಕಾರ ಉಪ ವಿಭಾಗಾಧಿಕಾರಿಗಳು, ಬಿಜಾಪುರ ಇವರು ಹೊರತುಪಡಿಸಿ ಐತೀರ್ಪಿನಂತೆ ಧನದ ಮೊತ್ತ ರೂ. 23,88,534-00 ಗಳನ್ನು (ಇಪ್ಪತ್ತ್ಮೂರು ಲಕ್ಷದ ಎಂಭತ್ತೆಂಟು ಸಾವಿರದ ಐನೂರ ಮೂವತ್ತ್ನಾಕು ರೂ.ಗಳು ಮಾತ್ರ). ಪ್ರಸ್ತಾವನೆಯಲ್ಲಿ ತಿಳಿಸಿರುವ ಸ.ನಂ.ಗಳಿಗೆ ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು. ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011-12ನೇ ಸಾಲಿನ ಆಯವ್ಯಯಕ್ಕಿಂತ ಲೆಕ್ಕಶೀರ್ಷಿಕೆ "4702-00-800-1-00 ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು-ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 23,88,534/-ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ:20-10-2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ.ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಪಿಆರ್ ನಂ. 1126 ಜಲಸಂಪನ್ಮೂಲ ಇಲಾಖೆ. (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಕೊಪ್ಪಳ ಜಿಲ್ಲೆ ಗಂಗಾವತಿ ತಾಲ್ಲೂಕಿನ ಇಂಗಳದಾಳ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ :** 1. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ: 29-07-2011ರ ಪತ್ರ ಸಂಖ್ಯೆ: ಮುಇಂ/ಸನೀ(ಉ)/ಭೂಸ್ವಾಪ್ರ/2011-12/4021.

**ಪ್ರಸ್ತಾವನೆ :**

ಕೊಪ್ಪಳ ಜಿಲ್ಲೆ. ಗಂಗಾವತಿ ತಾಲ್ಲೂಕಿನ ಇಂಗಳದಾಳ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಇಂಗಳದಾಳ ಗ್ರಾಮದ ಜಮೀನುಗಳಿಗೆ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ಕೊಪ್ಪಳ ಇವರು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ ಓದಲಾದ ದಿನಾಂಕ: 29-07-2011ರ ಪತ್ರದಲ್ಲಿ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 18-06-1987.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ: 22-09-1990.

ಗಂಗಾವತಿ ತಾಲ್ಲೂಕಿನ ಇಂಗಳದಾಳ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳ ಭೂಮಾಲೀಕರು ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ದಾಖಲಿಸಿದ್ದ ಎಲ್.ಎ.ಸಿ. ಪ್ರಕರಣಗಳಲ್ಲಿ ಕೊಪ್ಪಳದ ಸಿವಿಲ್ ಜಡ್ಜ್ ನ್ಯಾಯಾಲಯವು ಭೂಸ್ವಾಧೀನಾಧಿಕಾರಿಗಳು ಪ್ರತಿ ಎಕರೆಗೆ ನಿಗದಿಪಡಿಸಿದ್ದ ರೂ. 3,000/- ಗಳಿಂದ ರೂ. 11,500/- ಗಳಿಗೆ ಹೆಚ್ಚಿಸಿ ತೀರ್ಪು ನೀಡಿದೆ. ಈ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಇಲಾಖೆಯು ಪತ್ರ ಸಂಖ್ಯೆ: ಲಾ 452 ಎಲ್‌ಎಸ್‌ಜೆ 93, ದಿನಾಂಕ: 01-02-1993 ರಂದು ಅಭಿಪ್ರಾಯ ನೀಡಿದೆ. ಆದರೆ, ಭೂಮಾಲೀಕರು ಈ ತೀರ್ಪಿನಿಂದ ತೃಪ್ತರಾಗದೇ ಎಲ್.ಎ.ಸಿ. 179, 180, 184, 188, 200, 179, 172/91 ಮತ್ತು 201/91ರ ತೀರ್ಪುಗಳ ಮೇಲೆ ಕೊಪ್ಪಳದ ಜಿಲ್ಲಾ ಮತ್ತು ಸೆಷನ್ಸ್ ನ್ಯಾಯಾಲಯದಲ್ಲಿ ಮೇಲ್ಮನವಿ ಕ್ರಮವಾಗಿ ಎಂ.ಎ. ಸಂಖ್ಯೆ: 8/00, 9/00, 5/00, 19,95, 7/00, 24/95 ಮತ್ತು 4/00 ಗಳನ್ನು ದಾಖಲಿಸಿದ್ದಾರೆ.

ಎಲ್.ಎ.ಸಿ. 167/91 ಮತ್ತು 191/91ರ ತೀರ್ಪಿನ ಮೇಲೆ ಉಚ್ಚ ನ್ಯಾಯಾಲಯದಲ್ಲಿ ಕ್ರಮವಾಗಿ ಎಂ.ಎಫ್.ಎ. 1143/93 ಮತ್ತು 1737/93ನ್ನು ದಾಖಲಿಸಿದ್ದು, ಈ ಮೇಲ್ಮನವಿಗಳಲ್ಲಿ ಮಾನ್ಯ ನ್ಯಾಯಾಲಯವು ಪ್ರತಿ ಎಕರೆಗೆ ರೂ. 15,600/-ಗಳನ್ನು ನಿಗದಿಪಡಿಸಿದೆ. ಎಂ.ಎಫ್.ಎ. ಸಂಖ್ಯೆ: 1143/93ರ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು ಇಲಾಖೆಯು ಪತ್ರ ಸಂಖ್ಯೆ: ಲಾ 452 ಎಲ್‌ಸಿಜಿ 93, ದಿನಾಂಕ: 16-03-1996 ರಂದು ಅಭಿಪ್ರಾಯ ನೀಡಿದೆ.

ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ. ಸಂ. | ಎಲ್.ಎ.ಸಿ. | ಎಂ.ಎ. | ಇಂಗಳದಾಳ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂಪು | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|
| 1 | 179/91 | 8/2000 | 34/ಸಿ | 0–09 | 4849 |
| 2 | 180/91 | 9/2000 | 28/ಬಿ | 0–11 | 5815 |
| 3 | 184/91 | 5/2000 | 18.21 | 1–13 | 26100 |
| 4 | 188/91 | 19/95 | 5 | 1–30 | 34309 |
| 5 | 200/91 | 7/2000 | 27/1 | 0–23 | 11610 |
| 6 | 170/91 | 24/95 | 3/ಎ | 0–12 | 6296 |
| 7 | 172/91 | 11/95 | 5 | 1–36 | 37205 |
| 8 | 167/91 | 1143/91 | 13/1 | 2–02 | 40103 |
| 9 | 201/91 | 4/2000 | 35/ಎ | 0–04 | 2432 |
| 10 | 191/91 | 1737/93 | 5 | 2–04 | 41069 |
| | | | ಒಟ್ಟು | | **209788** |

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 99 ಭೂಸ್ವಾಪ್ರ 2011 ಬೆಂಗಳೂರು, ದಿನಾಂಕ: 31ನೇ ಮಾರ್ಚ್ 2012**

ಕೊಪ್ಪಳ ಜಿಲ್ಲೆ ಗಂಗಾವತಿ ತಾಲ್ಲೂಕಿನ ಇಂಗಳದಾಳ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಇಂಗಳದಾಳ ಗ್ರಾಮದ ಮೇಲ್ಕಂಡ ಸರ್ವೆ ನಂಬರ್ ಜಮೀನಗಳಿಗೆ ನ್ಯಾಯಾಲಯವು ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರ ಮೊತ್ತ ರೂ. 2,09,788–00ಗಳನ್ನು (ಎರಡು ಲಕ್ಷದ ಒಂಭತ್ತು ಸಾವಿರದ ಏಳುನೂರ ಎಂಭತ್ತೆಂಟು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು. ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2010–11ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00 ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು– ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 2,09,788/– ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ : 20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರಿದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ

**ಕೆ.ಸಿ.ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಪಿಆರ್ ನಂ. 1127 ಜಲಸಂಪನ್ಮೂಲ ಇಲಾಖೆ. (ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಗುಲ್ಬರ್ಗಾ ಜಿಲ್ಲೆ ಚಿಂಚೋಳಿ ತಾಲ್ಲೂಕು ಸಾಲೇಬೀರನಹಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ಸಮಿತಿ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ :** 1. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ: ಮುಇಂ/ಸನೀ(ಉ)/ವ/ಬಿಜಾ/–ಭೂಸ್ವಾಪ್ರ/2011–12/5584, ದಿನಾಂಕ: 02–11–2011.

**ಪ್ರಸ್ತಾವನೆ :**

ಗುಲ್ಬರ್ಗಾ ಜಿಲ್ಲೆ, ಚಿಂಚೋಳಿ ತಾಲ್ಲೂಕು ಸಾಲೇಬೀರನಹಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣದಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 05–04–2007.

- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧಿನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ: 12-11-2008.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಚಿಂಚೋಳಿ ಸಿವಿಲ್ (ಹಿರಿಯ ವಿಭಾಗ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣಗಳನ್ನು ದಾಖಲಿಸಿದ್ದು, ನ್ಯಾಯಾಲಯವು ಎಲ್.ಎ.ಸಿ. ಸಂಖ್ಯೆ: 64/07, ದಿನಾಂಕ: 19-02-2010, ಎಲ್.ಎ.ಸಿ. 67/09, ದಿನಾಂಕ: 06-02-2009, ಎಲ್.ಎ.ಸಿ. 61/09, ದಿನಾಂಕ: 09-02-2010 ಹಾಗೂ ಎಲ್.ಎ.ಸಿ. 55/09, ದಿನಾಂಕ: 23-06-2010 ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ಜಮೀನಿಗೆ ರೂ. 1,57,000/-ಗಳ ಭೂಮೌಲ್ಯವನ್ನು ನಿಗದಿಪಡಿಸಿ ಇತರೆ ಸವಲತ್ತುಗಳೊಂದಿಗೆ ಪಾವತಿಸಲು ಆದೇಶಿಸಿದೆ. ಈ ಆದೇಶಗಳ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು ಇಲಾಖೆಯು ಪತ್ರ ಸಂಖ್ಯೆ: ಆರ್‌ಡಿ 1130 ಎಲ್‌ಸಿಜಿ 10, ಆರ್‌ಡಿ 1131 ಎಲ್‌ಸಿಜಿ 10, ಆರ್‌ಡಿ 1148 ಎಲ್‌ಸಿಜಿ 10, ಆರ್‌ಡಿ 1133 ಎಲ್‌ಸಿಜಿ 10 ಮತ್ತು ಆರ್‌ಡಿ 112 ಎಲ್‌ಸಿಜಿ 10, ದಿನಾಂಕ: 31-12-19ರ ಪತ್ರಗಳಲ್ಲಿ ಅಭಿಪ್ರಾಯ ನೀಡಿದೆ ಪಾವತಿಸಬೇಕಾದ ಪರಿಹಾರದ ವಿವರ ಕೆಳಕಂಡಂತಿದೆ:

| ಕ್ರಮ ಸಂಖ್ಯೆ | ಎಲ್.ಎ.ಸಿ ಸಂಖ್ಯೆ | ಸಾಲೇಬೀರನಹಳ್ಳಿ ಗ್ರಾಮದ ಸ.ನಂ. | ವಿಸ್ತೀರ್ಣ ಎ-ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|
| 1 | 64/09 | 20/ಬಿ | 0-20 | 125091 |
| 2 | 67/09 | 27/5 | 0-20 | 125091 |
| 3 | 61/09 | 17/1 | 1-00 | 243836 |
| 4 | 132/09 | 3/1, 3/2 | 2-14 | 586816 |
| 5 | 55/09 | 16/1 | 2-27 | 667929 |
| | ಒಟ್ಟು | | | **1748763** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ, ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 157 ಭೂಸ್ವಾಪ್ರ 2011 ಬೆಂಗಳೂರು, ದಿನಾಂಕ: 30ನೇ ಮಾರ್ಚ್ 2012**

ಗುಲ್ಬರ್ಗಾ ಜಿಲ್ಲೆ, ಚಿಂಚೋಳಿ ತಾಲ್ಲೂಕು ಸಾಲೇಬೀರನಹಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಸಾಲೇಬೀರನಹಳ್ಳಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸ.ನಂ.ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ. 17,48,763/-ಗಳನ್ನು (ಹದಿನೇಳು ಲಕ್ಷದ ನಲವತ್ತೆಂಟು ಸಾವಿರದ ಏಳುನೂರ ಅರವತ್ಮೂರು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು. ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011-12ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702-00-800-1-00 ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು-ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 17,48,763/-ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ:20-10-2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ. (ಸಣ್ಣ ನೀರಾವರಿ)

ಪಿಆರ್ ನಂ. 1128

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಗುಲ್ಬರ್ಗಾ ಜಿಲ್ಲೆ ಚಿಂಚೋಳಿ ತಾಲ್ಲೂಕು ಸಾಲೇಬೀರನಹಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ :** 1. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ: ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011-12/5726, ದಿನಾಂಕ : 10-11-2011.

**ಪ್ರಸ್ತಾವನೆ :**

ಗುಲ್ಬರ್ಗಾ ಜಿಲ್ಲೆ, ಚಿಂಚೋಳಿ ತಾಲ್ಲೂಕು ಸಾಲೇನೀರನಹಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಲ್ಕೊಳ್ಳಲಾದ ಸಾಲೇಬೀರನಹಳ್ಳಿ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣದಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

– ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 19–11–1992.
– ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ: 22–09–1995.

ಭೂಸ್ವಾಧೀನಾಧಿಕಾರಿಗಳಾದ ಐತೀರ್ಪಿನಂತೆ ಪರಿಹಾರ ಧನ ಪಡೆದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಚಿಂಚೋಳಿ ಸಿವಿಲ್ (ಹಿರಿಯ ವಿಭಾಗ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣ ಸಂಖ್ಯೆ: 714/97ನ್ನು ದಾಖಲಿಸಿದ್ದು, ನ್ಯಾಯಾಲಯವು ದಿನಾಂಕ: 19–12–1999 ರಂದು ನೀಡಿದ ಸಾಮಾನ್ಯ ಆದೇಶದಲ್ಲಿ ಪ್ರತಿ ಎಕರೆ ರೂ. 26,000/–ಗಳನ್ನು ನಿಗದಿಪಡಿಸಿ ಇತರೆ ಸವಲತ್ತುಗಳೊಂದಿಗೆ ಪಾವತಿಸಲು ದಿನಾಂಕ: 13–11–2009 ರಂದು ಆದೇಶಿಸಿದೆ. ಇದಕ್ಕೆ ತೃಪ್ತರಾಗದ ಭೂಮಾಲೀಕರು ಉಚ್ಚ ನ್ಯಾಯಾಲಯದಲ್ಲಿ ಎಂ.ಎಸ್.ಎ. ಸಂಖ್ಯೆ: 97/07ನ್ನು ದಾಖಲಿಸಿದ್ದು, ಉಚ್ಚ ನ್ಯಾಯಾಲಯವು ಭೂಮೌಲ್ಯವನ್ನು ರೂ. 36,790/– ಗಳಿಗೆ ಹೆಚ್ಚಿಸಿ ತೀರ್ಪು ನೀಡಿದೆ. ಈ ತೀರ್ಪನ್ನು ಸಹ ಒಪ್ಪದ ಭೂಮಾಲೀಕರು ಸರ್ವೋಚ್ಚ ನ್ಯಾಯಾಲಯದಲ್ಲಿ ಎಸ್.ಎಲ್.ಪಿ. ಸಂಖ್ಯೆ: 31001/08ನ್ನು ದಾಖಲಿಸಿದ್ದು, ಮಾನ್ಯ ಸರ್ವೋಚ್ಚ ನ್ಯಾಯಾಲಯವು ದಿನಾಂಕ: 31–01–2011 ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆಗೆ ರೂ. 61,310/–ಗಳನ್ನು ನಿಗದಿಪಡಿಸಿದೆ. ನ್ಯಾಯಾಲಯವು ಹೆಚ್ಚಿನ ಪರಿಹಾರಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ

| ಕ್ರ. ಸಂ. | ಎಲ್.ಎ.ಸಿ. ಸಂಖ್ಯೆ | ಎಂ.ಎಸ್.ಎ | ಎಸ್ಎಲ್‌ಪಿ | ಸಾಲೇಬೀರನಹಳ್ಳಿ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|---|
| 1 | 714/97 | 97/07 | 31001/08 | 152/2ಸಿ, 18/ID | 7–34 | 10,25,289–00 |
| | ಒಟ್ಟು | | | | | **10,25,289–00** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ, ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 164 ಭೂಸ್ವಾಪ್ರ 2011 ಬೆಂಗಳೂರು, ದಿನಾಂಕ: 30ನೇ ಮಾರ್ಚ್ 2012**

ಗುಲ್ಬರ್ಗಾ ಜಿಲ್ಲೆ, ಚಿಂಚೋಳಿ ತಾಲ್ಲೂಕು ಸಾಲೇಬೀರನಹಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಸಾಲೇಬೀರನಹಳ್ಳಿ ಗ್ರಾಮಕ್ಕೆ ಸೇರಿದ 152/2ಸಿ, 18/1ಡಿ ರ ಜಮೀನುಗಳಿಗೆ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ. 10,25,289/–ಗಳನ್ನು (ಹತ್ತು ಲಕ್ಷದ ಇಪ್ಪತ್ತೈದು ಸಾವಿರದ ಇನ್ನೂರ ಎಂಭತ್ತೊಂಭತ್ತು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು. ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2011–12ನೇ ಸಾಲಿನ ಆಯವ್ಯಯಕ್ಕಿಂತ ಲೆಕ್ಕಶೀರ್ಷಿಕೆ "4702–00–800–1–00 ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಮರುಹೊಂದಾಣಿಕೆ ಅನುದಾನದಿಂದ ರೂ. 10,25,289/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ:20–10–2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ. (ಸಣ್ಣ ನೀರಾವರಿ)

ಪಿಆರ್ ನಂ. 1129

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಓಕಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ :** 1. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ: ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011-12/734, ದಿನಾಂಕ: 18–02–2012.

**ಪ್ರಸ್ತಾವನೆ :**

ಗುಲ್ಬರ್ಗಾ ಜಿಲ್ಲೆ, ಮತ್ತು ತಾಲ್ಲೂಕು ಓಕಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಓಕಳಿ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣದಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

